**ವಿದ್ಯಾರ್ಹತೆಃ**

| ಶೀಘ್ರಲಿಪಿಗಾರರು | ಬೆರಳಚ್ಚುಗಾರರು |
|---|---|
| 1. ಎಸ್.ಎಸ್.ಎಲ್.ಸಿ. ಅಥವಾ ತತ್ಸಮಾನ ಪರೀಕ್ಷೆಯಲ್ಲಿ ಉತ್ತೀರ್ಣರಾಗಿರಬೇಕು.<br>2. ಕರ್ನಾಟಕ ಪ್ರೌಢ ಶಿಕ್ಷಣ ಪರೀಕ್ಷಾ ಮಂಡಳಿಯವರು ನಡೆಸುವ ಕನ್ನಡ ಮತ್ತು ಆಂಗ್ಲ ಪ್ರೌಢದರ್ಜೆ (Senior Grade) ಶೀಘ್ರಲಿಪಿ ಹಾಗೂ ಕನ್ನಡ ಮತ್ತು ಆಂಗ್ಲ ಬೆರಳಚ್ಚು ಪ್ರೌಢದರ್ಜೆ ಪರೀಕ್ಷೆ ಅಥವಾ ತತ್ಸಮಾನ ಪರೀಕ್ಷೆಯಲ್ಲಿ ಉತ್ತೀರ್ಣರಾಗಿರಬೇಕು.<br>3. ಕಂಪ್ಯೂಟರ್ ಶಿಕ್ಷಣದ ಅರ್ಹತೆ ಅಗತ್ಯ (ಅರ್ಹತಾ ಪತ್ರಗಳನ್ನು ಖಡ್ಡಾಯವಾಗಿ ಲಗತ್ತಿಸತಕ್ಕದ್ದು) | 1. ಎಸ್.ಎಸ್.ಎಲ್.ಸಿ. ಅಥವಾ ತತ್ಸಮಾನ ಪರೀಕ್ಷೆಯಲ್ಲಿ ಉತ್ತೀರ್ಣರಾಗಿರಬೇಕು.<br>2. ಕರ್ನಾಟಕ ಪ್ರೌಢ ಶಿಕ್ಷಣ ಪರೀಕ್ಷಾ ಮಂಡಳಿಯವರು ನಡೆಸುವ ಕನ್ನಡ ಮತ್ತು ಆಂಗ್ಲ ಬೆರಳಚ್ಚು ಪ್ರೌಢದರ್ಜೆ (Senior Grade) ಪರೀಕ್ಷೆ ಅಥವಾ ತತ್ಸಮಾನ ಪರೀಕ್ಷೆಯಲ್ಲಿ ಉತ್ತೀರ್ಣರಾಗಿರಬೇಕು.<br>3. ಕಂಪ್ಯೂಟರ್ ಶಿಕ್ಷಣದ ಅರ್ಹತೆ ಅಗತ್ಯ (ಅರ್ಹತಾ ಪತ್ರಗಳನ್ನು ಖಡ್ಡಾಯವಾಗಿ ಲಗತ್ತಿಸತಕ್ಕದ್ದು) |

**ಅರ್ಜಿಯಲ್ಲಿ ಮೀಸಲಾತಿಗೆ ಸಂಬಂಧಿಸಿದ ಅಂಕಣದಲ್ಲಿ ಉಪಯೋಗಿಸಿದ ಸಂಕ್ಷಿಪ್ತ ಪದಗಳ ಅರ್ಥವನ್ನು ಈ ಕೆಳಕಂಡಂತೆ ಅರ್ಥೈಸಿಕೊಳ್ಳಬೇಕು.**

| | |
|---|---|
| ಸಾ.ಅ. – ಸಾಮಾನ್ಯ ಅಭ್ಯರ್ಥಿ | ಪ.ಜಾ. – ಪರಿಶಿಷ್ಟ ಜಾತಿ |
| ಪ.ಪಂ. – ಪರಿಶಿಷ್ಟ ಪಂಗಡ | ಪ್ರ.1 – ಪ್ರವರ್ಗ 1 |
| ಮ.ಅ. – ಮಹಿಳಾ ಅಭ್ಯರ್ಥಿ | ಗ್ರಾ.ಅ. – ಗ್ರಾಮೀಣ ಅಭ್ಯರ್ಥಿ |
| ಕ.ಮಾ.ಅ. – ಕನ್ನಡ ಮಾಧ್ಯಮ ಅಭ್ಯರ್ಥಿ | ಅಂ.ಅ. – ಅಂಗವಿಕಲ ಅಭ್ಯರ್ಥಿ |
| ಮಾ.ಸೈ.ಅ. – ಮಾಜಿ ಸೈನಿಕ ಅಭ್ಯರ್ಥಿ | ಯೋ.ನಿ.ಅ. – ಯೋಜನಾ ನಿರಾಶ್ರಿತ ಅಭ್ಯರ್ಥಿ |

**ಃ ವಯೋಮಿತಿ (ಅರ್ಜಿ ಸಲ್ಲಿಸಲು ಕೊನೆಯ ದಿನಾಂಕಕ್ಕೆ ಅನುಗುಣವಾಗಿ) ಃ**

**ಕನಿಷ್ಠ ವಯೋಮಿತಿ : 18 ವರ್ಷ**

**ಗರಿಷ್ಠ ವಯೋಮಿತಿ : ಸಾಮಾನ್ಯ ವರ್ಗ – 35 ವರ್ಷ**

2ಎ /2ಬಿ /3ಎ /3ಬಿ – 38 ವರ್ಷ

ಪ.ಜಾ/ಪ.ಪಂ/ಪ್ರವರ್ಗ – 40 ವರ್ಷ

ಸರ್ಕಾರಿ ಸೇವೆಯಲ್ಲಿರುವವರಿಗೆ, ವಿಧವೆಯರಿಗೆ, ಮಾಜಿ ಸೈನಿಕರಿಗೆ ಹಾಗೂ ಅಂಗವಿಕಲರಿಗೆ ನಿಯಮಾನುಸಾರ ವಯೋಮಿತಿಯಲ್ಲಿ ಸಡಿಲಿಕೆ ನೀಡಲಾಗುವುದು.

**ವೇತನ ಶ್ರೇಣಿಃ**

**ಶೀಘ್ರಲಿಪಿಗಾರರು :** 14550–350–15600–400–17200–450–19000–500–21000–600–24600–700–26700 ಮತ್ತು ಇತರೆ ಭತ್ಯೆಗಳು.

**ಬೆರಳಚ್ಚುಗಾರರು :** 11600–200–12000–250–13000–300–14200–350–15600–400–17200–450–19000–500–21000 ಮತ್ತು ಇತರೆ ಭತ್ಯೆಗಳು.

**ಆಯ್ಕೆ ವಿಧಾನಃ**

ಕರ್ನಾಟಕ ಅಧೀನ ನ್ಯಾಯಾಲಯಗಳು (ಮಿನಿಸ್ಟ್ರಿಯಲ್ ಮತ್ತು ಇತರೆ ಹುದ್ದೆಗಳು) (ನೇಮಕಾತಿ) (ತಿದ್ದುಪಡಿ) ನಿಯಮಗಳು 2007 ರ ಅನ್ವಯ ನೇರ ನೇಮಕಾತಿಯ ಮೂಲಕ ಆಯ್ಕೆ ಮಾಡಲಾಗುವುದು.

**1. ಶೀಘ್ರಲಿಪಿಗಾರರುಃ**

ಅರ್ಹತಾ ಪರೀಕ್ಷೆಗಳಲ್ಲಿ ಗಳಿಸಿರುವ ಒಟ್ಟು ಶೇಕಡಾವಾರು ಅಂಕಗಳು ಮತ್ತು ನಿಮಿಷ 1ಕ್ಕೆ 120 ಪದಗಳ ದರದಲ್ಲಿ 5 ನಿಮಿಷಗಳ ಉಕ್ತಲೇಖನವನ್ನು ತೆಗೆದುಕೊಂಡು ಉಕ್ತಲೇಖನವನ್ನು 40 ನಿಮಿಷಗಳಲ್ಲಿ ಅನುಲಿಪಿ ಮಾಡುವ ಅರ್ಹತಾ ಪರೀಕ್ಷೆಯಲ್ಲಿ ಗಳಿಸುವ ಅಂಕಗಳು ಮತ್ತು ಸಂದರ್ಶನದಲ್ಲಿ ಗಳಿಸುವ ಅಂಕಗಳ ಆಧಾರದ ಮೇಲೆ ಆಯ್ಕೆ ಮಾಡಲಾಗುವುದು. 1 ಹುದ್ದೆಗೆ 5 ಅಭ್ಯರ್ಥಿಗಳಂತೆ ಅತಿ ಹೆಚ್ಚು ಅಂಕ ಪಡೆದ ಅಭ್ಯರ್ಥಿಗಳನ್ನು ಸಂದರ್ಶನಕ್ಕೆ ಕರೆಯಲಾಗುವುದು. (1ಃ5 ರ ಅನುಪಾತದಲ್ಲಿ)

**ಟಿಪ್ಪಣಿಃ** ಅರ್ಹತಾ ಪರೀಕ್ಷೆಯಲ್ಲಿ ಗರಿಷ್ಠ 100 ಅಂಕಗಳನ್ನು ಪಡೆದಿದ್ದು ಅದರಲ್ಲಿ ತೇರ್ಗಡೆಯಾಗಲು ಕನಿಷ್ಠ 50 ಅಂಕಗಳನ್ನು ಪಡೆಯಬೇಕು ಮತ್ತು ಸಂದರ್ಶನವು 5 ಅಂಕಗಳನ್ನು ಒಳಗೊಂಡಿರುತ್ತದೆ.

**2. ಬೆರಳಚ್ಚುಗಾರರು :**

ಅರ್ಹತಾ ಪರೀಕ್ಷೆಗಳಲ್ಲಿ ಗಳಿಸಿರುವ ಒಟ್ಟು ಶೇಕಡಾವಾರು ಅಂಕಗಳು ಮತ್ತು 15 ನಿಮಿಷಗಳ ಉಕ್ತಲೇಖನದಲ್ಲಿ ಕೊಡುವ ವಿಷಯವನ್ನು ಬೆರಳಚ್ಚು ಮಾಡುವ ಅರ್ಹತಾ ಪರೀಕ್ಷೆಯಲ್ಲಿ ಗಳಿಸುವ ಅಂಕಗಳು ಮತ್ತು ಸಂದರ್ಶನದಲ್ಲಿ ಗಳಿಸುವ ಅಂಕಗಳ ಆಧಾರದ ಮೇಲೆ ಆಯ್ಕೆ ಮಾಡಲಾಗುವುದು. 1 ಹುದ್ದೆಗೆ 5 ಅಭ್ಯರ್ಥಿಗಳಂತೆ ಅತಿ ಹೆಚ್ಚು ಅಂಕ ಪಡೆದ ಅಭ್ಯರ್ಥಿಗಳನ್ನು ಸಂದರ್ಶನಕ್ಕೆ ಕರೆಯಲಾಗುವುದು. (1:5 ರ ಅನುಪಾತದಲ್ಲಿ)

**ಟಿಪ್ಪಣಿ:** ಅರ್ಹತಾ ಪರೀಕ್ಷೆಯಲ್ಲಿ ಗರಿಷ್ಠ 100 ಅಂಕಗಳನ್ನು ಒಳಗೊಂಡಿದ್ದು, ಅದರಲ್ಲಿ ತೇರ್ಗಡೆಯಾಗಲು ಕನಿಷ್ಠ 50 ಅಂಕಗಳನ್ನು ಪಡೆಯಬೇಕು. ಮತ್ತು ಸಂದರ್ಶನವು 5 ಅಂಕಗಳನ್ನು ಒಳಗೊಂಡಿರುತ್ತದೆ.

**ಟಿಪ್ಪಣಿ: ಸಂದರ್ಶನವು 10 ಅಂಕಗಳನ್ನು ಒಳಗೊಂಡಿರುತ್ತದೆ.**

ಅಭ್ಯರ್ಥಿಗಳನ್ನು 2 ವರ್ಷಗಳ ಕಾಲ ಪರೀಕ್ಷಣಾ ಅವಧಿಯಲ್ಲಿಡಲಾಗುವುದು.

**ಲಗತ್ತಿಸಬೇಕಾದ ದಾಖಲಾತಿಗಳು:**

**ಅಭ್ಯರ್ಥಿಗಳು ಈ ಕೆಳಕಂಡ ಪ್ರಮಾಣಪತ್ರಗಳ ಒಂದೊಂದು ಫೋಟೋ ಪ್ರತಿಗಳನ್ನು (Xerox Copy) ಸ್ವಯಂ ದೃಢೀಕರಿಸಿ ಅರ್ಜಿಯೊಂದಿಗೆ ಲಗತ್ತಿಸಬೇಕು. ಕೊನೆಯ ದಿನಾಂಕದ ನಂತರ ಸಲ್ಲಿಸಲಾದ ಯಾವುದೇ ಅರ್ಜಿಗಳನ್ನು ಪರಿಗಣಿಸಲಾಗುವುದಿಲ್ಲ.**

1. ಹುದ್ದೆಗಳಿಗೆ ನಿಗದಿಪಡಿಸಲಾದ ವಿದ್ಯಾರ್ಹತೆಯ ಅಂಕಪಟ್ಟಿಗಳು ಹಾಗೂ ಪ್ರಮಾಣಪತ್ರಗಳು.
2. ಜನ್ಮದಿನಾಂಕವನ್ನು ನಮೂದಿಸಿರುವ ಎಸ್.ಎಸ್.ಎಲ್.ಸಿ. ಅಥವಾ ತತ್ಸಮಾನ / ಕಂಪ್ಯೂಟರ್ ಶಿಕ್ಷಣದ ಅರ್ಹತಾ ಪರೀಕ್ಷೆಯ ಪ್ರಮಾಣ ಪತ್ರ, ವರ್ಗಾವಣೆ ಪ್ರಮಾಣಪತ್ರ, / ಜನ್ಮ ದಿನಾಂಕವನ್ನು ತೋರಿಸುವ ಸಂಚಿತ ದಾಖಲೆಯ ಉದ್ಧೃತ ಭಾಗ
3. ಸೈನಿಕ ಸೇವೆಯಿಂದ ಬಿಡುಗಡೆಯಾದ /ಮುಕ್ತಿಹೊಂದಿದ ಬಗ್ಗೆ ಪ್ರಮಾಣಪತ್ರ. (ಮಾಜಿಸೈನಿಕ ಮೀಸಲಾತಿ ಕೋರಿದ್ದಲ್ಲಿ)
4. ಪರಿಶಿಷ್ಠ ಜಾತಿ/ಪರಿಶಿಷ್ಟ ಪಂಗಡ ನಮೂನೆ –ಡಿ ಯಲ್ಲಿ, ಪ್ರವರ್ಗ–1 ರ ಅಭ್ಯರ್ಥಿಗಳು ನಮೂನೆ–ಇ ಯಲ್ಲಿ ಮತ್ತು 2–ಎ, 2–ಬಿ, 3–ಎ, 3–ಬಿ ಅಭ್ಯರ್ಥಿಗಳು ನಮೂನೆ ಎಫ್ ರಲ್ಲಿ ಸಂಬಂಧಿಸಿದ ತಹಸೀಲ್ದಾರರಿಂದ ಜಾತಿ ಮತ್ತು ಆದಾಯ ಪ್ರಮಾಣಪತ್ರಗಳನ್ನು ಪಡೆದು ಲಗತ್ತಿಸಬೇಕು.
5. ಶಾಲಾ ಮುಖ್ಯೋಪಾಧ್ಯಾಯರು/ ಪ್ರಾಂಶುಪಾಲರಿಂದ ಪಡೆದ ಒಂದು ನಡತೆ ಪ್ರಮಾಣ ಪತ್ರ ಹಾಗೂ ಸ್ಥಳೀಯ ಗಣ್ಯ ವ್ಯಕ್ತಿಗಳಿಂದ ಪಡೆದ ಎರಡು ನಡತೆ ಪ್ರಮಾಣ ಪತ್ರಗಳು.
6. ಗ್ರಾಮೀಣ ಮೀಸಲಾತಿಯನ್ನು ಕೋರುವ ಅಭ್ಯರ್ಥಿಗಳು ಸರ್ಕಾರಿ ಆದೇಶ ಸಂಖ್ಯೆ:ಸಿಆಸುಇ/96/ಸೇನನಿ/2005ದ ದಿನಾಂಕ: 10.08.2005 ರ ಪ್ರಕಾರ ನಿಗದಿತ ನಮೂನೆ–2 ರಲ್ಲಿ ಅಧಿಕೃತ ಅಧಿಕಾರಿಗಳಿಂದ ಪಡೆದು ಅದನ್ನು ಸಂಬಂಧಿಸಿದ ಕ್ಷೇತ್ರ ಶಿಕ್ಷಣಾಧಿಕಾರಿಗಳಿಂದ ಮೇಲು ಸಹಿ ಮಾಡಿಸಿ ಸಲ್ಲಿಸಬೇಕು. ಗ್ರಾಮೀಣ ಮೀಸಲಾತಿ ಕೋರುವ ಪರಿಶಿಷ್ಟ ಜಾತಿ, ಪರಿಶಿಷ್ಟ ಪಂಗಡ ಹಾಗೂ ಹಿಂದುಳಿದ ವರ್ಗಗಳಿಗೆ ಸೇರಿದ ಅಭ್ಯರ್ಥಿಗಳ ಮೀಸಲಾತಿ ಪ್ರಮಾಣ ಪತ್ರಗಳು ತಿರಸ್ಕೃತಗೊಂಡಲ್ಲಿ ಅವರು ಗ್ರಾಮೀಣ ಮೀಸಲಾತಿಗೂ ಅನರ್ಹರಾಗುತ್ತಾರೆ.
7. ಗ್ರಾಮೀಣ ಮೀಸಲಾತಿಯನ್ನು ಕೋರುವ ಸಾಮಾನ್ಯ ವರ್ಗದ ಅಭ್ಯರ್ಥಿಗಳು ಪ್ರಮಾಣಪತ್ರ ನಮೂನೆ–2 ರ ಜೊತೆ ನಮೂನೆ–1 ರಲ್ಲೂ ದೃಢೀಕರಣ ಪತ್ರವನ್ನು ಸಲ್ಲಿಸುವುದು.
8. ವಿಧವೆಯರು, ಜೀತ ಕಾರ್ಮಿಕರು ಹಾಗೂ ವಯೋಮಿತಿ ರಿಯಾಯಿತಿಗೆ ಅರ್ಹರಾದ ಇನ್ನಿತರರು ವಯೋಮಿತಿ ರಿಯಾಯಿತಿ ಕೋರಲು ಸಕ್ಷಮ ಪ್ರಾಧಿಕಾರದಿಂದ ಪಡೆದ ಪ್ರಮಾಣಪತ್ರವನ್ನು ಸಲ್ಲಿಸುವುದು.
9. ಅರ್ಹತಾ ಪರೀಕ್ಷೆಗೆ ಹಾಜರಾಗುವ ಅಭ್ಯರ್ಥಿಗಳು ತಮ್ಮ ಸ್ವಂತ ಖರ್ಚಿನಲ್ಲಿ ಹಾಜರಾಗುವುದು.

**ಪ್ರಮುಖವಾದ ಸೂಚನೆಗಳು:**

ಈ ಕೆಳಗಿನ ಸಂಧರ್ಭಗಳಲ್ಲಿ ನೇಮಕಾತಿಯ ಗರಿಷ್ಠ ವಯೋಮಿತಿಯನ್ನು ಆಯಾ ಅಭ್ಯರ್ಥಿಗಳಿಗೆ ನಮೂದಿಸಿರುವ ಮಟ್ಟಿಗೆ ಹೆಚ್ಚಿಸಲಾಗುವುದು.

1. ಅಭ್ಯರ್ಥಿಯು ಕರ್ನಾಟಕ ರಾಜ್ಯ ಸರ್ಕಾರದಲ್ಲಿ ಅಥವಾ ಸ್ಥಳೀಯ ಪ್ರಾಧಿಕಾರದಲ್ಲಿ ಅಥವಾ ರಾಜ್ಯ ಅಧಿನಿಯಮ ಅಥವಾ ಕೇಂದ್ರ ಅಧಿನಿಯಮದ ಮೂಲಕ ಸ್ಥಾಪನೆಯಾದ ಅಥವಾ ರಾಜ್ಯ ಅಧಿನಿಯಮ ಅಥವಾ ರಾಜ್ಯ ಅಧಿನಿಯಮ ಅಥವಾ ಕೇಂದ್ರ ಅಧಿನಿಯಮದ ಮೂಲಕ ಸ್ಥಾಪನೆಗೊಂಡು ಕರ್ನಾಟಕ ರಾಜ್ಯ ಸರ್ಕಾರದ ಸ್ವಾಮ್ಯ ಅಥವಾ ನಿಯಂತ್ರಣದಲ್ಲಿರುವ ನಿಗಮದಲ್ಲಿ ಹುದ್ದೆ ಹೊಂದಿರುವ ಅಥವಾ ಹಿಂದೆ ಹೊಂದಿದ್ದಲ್ಲಿ ಗರಿಷ್ಠ ವಯೋಮಿತಿಯನ್ನು ಅವರು ಎಷ್ಟು ವರ್ಷಗಳ ಅವಧಿಗೆ ಹುದ್ದೆಯಲ್ಲಿ ಸೇವೆ ಸಲ್ಲಿಸಿರುವರೋ ಅಥವಾ ಹಿಂದೆ ಸಲ್ಲಿಸಿದ್ದರೋ ಅಷ್ಟು ವರ್ಷಗಳು ಅಥವಾ 10 ವರ್ಷಗಳ ಅವಧಿ, ಎರಡರಲ್ಲಿ ಯಾವುದು ಕಡಿಮೆಯೋ ಅಷ್ಟು ವರ್ಷಗಳ ಸಡಿಲಿಕೆಯನ್ನು ನೀಡಲಾಗುವುದು.

2. ಅಭ್ಯರ್ಥಿಯು ಮಾಜಿ ಸೈನಿಕನಾಗಿದ್ದಲ್ಲಿ, ಅವನು ಸಶಸ್ತ್ರ ದಳಗಳಲ್ಲಿ ಎಷ್ಟು ವರ್ಷ ಸೇವೆ ಸಲ್ಲಿಸಿರುವನೋ ಆ ವರ್ಷಗಳಿಗೆ 03 ವರ್ಷಗಳನ್ನು ಸೇರಿಸಿದರೆ ಎಷ್ಟು ವರ್ಷಗಳಾಗುವುವೋ ಅಷ್ಟು ವರ್ಷಗಳು.
3. ಅಭ್ಯರ್ಥಿಯು ಅಂಗವಿಕಲನಾಗಿದ್ದಲ್ಲಿ, ವಿಧವೆಯಾಗಿದ್ದಲ್ಲಿ ಮತ್ತು ಜೀತ ಕಾರ್ಮಿಕನಾಗಿದ್ದಲ್ಲಿ 10 ವರ್ಷಗಳು.
4. ಅಭ್ಯರ್ಥಿಯು ಕರ್ನಾಟಕ ರಾಜ್ಯದಲ್ಲಿರುವ ಭಾರತ ಸರ್ಕಾರದ ಜನಗಣತಿ ಸಂಸ್ಥೆಯಲ್ಲಿ ಈಗ ಹುದ್ದೆಯನ್ನು ಹೊಂದಿದ್ದ ಪಕ್ಷದಲ್ಲಿ ಗರಿಷ್ಠ ವಯೋಮಿತಿಯನ್ನು ಅಭ್ಯರ್ಥಿಯು ಎಷ್ಟು ವರ್ಷಗಳ ಅವಧಿಗೆ ಆ ಹುದ್ದೆಯಲ್ಲಿ ಸೇವೆ ಸಲ್ಲಿಸುತ್ತಿರುವರೋ ಅಥವಾ ಹಿಂದೆ ಸೇವೆ ಸಲ್ಲಿಸಿದ್ದಾರೋ ಅಷ್ಟು ವರ್ಷಗಳ ಅಥವಾ 05 ವರ್ಷಗಳ ಅವಧಿ, ಅದರಲ್ಲಿ ಯಾವುದು ಕಡಿಮೆಯೋ ಅಷ್ಟು ವರ್ಷಗಳು.
5. **ಸೇವೆಯಲ್ಲಿರುವ ಅಭ್ಯರ್ಥಿಗಳು ಅರ್ಜಿಯೊಂದಿಗೆ ತಮ್ಮ ಮೇಲಾಧಿಕಾರಿಗಳಿಂದ ಪಡೆದ ನಿರಾಕ್ಷೇಪಣಾ ಪ್ರಮಾಣ ಪತ್ರವನ್ನು ಲಗತ್ತಿಸತಕ್ಕದ್ದು.**
6. ಅಭ್ಯರ್ಥಿಯು ನ್ಯಾಷನಲ್ ಕೆಡೆಟ್ ಕಾರ್ಪ್ಸ್‌ನಲ್ಲಿ ಪೂರ್ಣಕಾಲಿಕ ಪರೀಕ್ಷಕರಾಗಿ ಸೇವೆ ಸಲ್ಲಿಸಿ ಬಿಡುಗಡೆಯಾಗಿರುವ ವ್ಯಕ್ತಿಯಾಗಿದ್ದರೆ ಅಂತಹ ಕೆಡೆಟ್ ಪರೀಕ್ಷಕನಾಗಿ ಸೇವೆ ಸಲ್ಲಿಸಿದ್ದಷ್ಟು ವರ್ಷಗಳು.
7. ಅಭ್ಯರ್ಥಿಯು ರಾಜ್ಯ ಸರ್ಕಾರದಿಂದ ಪುರಸ್ಕೃತವಾದ ಗ್ರಾಮೀಣ ಔದ್ಯಮೀಕರಣ ಯೋಜನೆಯ ಮೇರೆಗೆ ನೇಮಕಗೊಂಡು ಗ್ರಾಮಸಮೂಹ ಪರಿಶೀಲಕರಾಗಿ ಈಗ ಕೆಲಸ ಮಾಡುತ್ತಿದ್ದರೆ ಅಥವಾ ಹಿಂದೆ ಇದ್ದ ಪಕ್ಷದಲ್ಲಿ ಅಂತಹ ಗ್ರಾಮ ಸಮೂಹ ಪರಿಶೀಲಕರಾಗಿ ಸೇವೆ ಸಲ್ಲಿಸಿದ್ದಷ್ಟು ವರ್ಷಗಳು.

**ಇತರೆ ಸೂಚನೆಗಳು:**

1. ಅರ್ಜಿಗಳನ್ನು ಸ್ವೀಕರಿಸಲು ನಿಗದಿಪಡಿಸಿದ ಕೊನೆಯ ದಿನಾಂಕವು ಸಾರ್ವತ್ರಿಕ ರಜಾ ದಿನವಾಗಿ ಘೋಷಿಸಲ್ಪಟ್ಟರೆ ಆ ದಿನಾಂಕದ ಮಾರನೆಯ ಕೆಲಸದ ದಿನವು ಅರ್ಜಿಗಳನ್ನು ಸ್ವೀಕರಿಸಲು ಕೊನೆಯ ದಿನಾಂಕವಾಗುವುದು.
2. ಒಂದಕ್ಕಿಂತ ಹೆಚ್ಚು ಹುದ್ದೆಗೆ ಅರ್ಜಿ ಸಲ್ಲಿಸುವವರು ಪ್ರತಿ ಹುದ್ದೆಗಳಿಗೂ ಪ್ರತ್ಯೇಕವಾಗಿ ಅರ್ಜಿಗಳನ್ನು ಸಲ್ಲಿಸತಕ್ಕದ್ದು.
3. ಅರ್ಜಿಯಲ್ಲಿ ಮತ್ತು ಲಕೋಟೆಯ ಮೇಲೆ ಹುದ್ದೆಯ ಹೆಸರನ್ನು ಕಡ್ಡಾಯವಾಗಿ ನಮೂದಿಸತಕ್ಕದ್ದು.
4. ಅರ್ಜಿಯೊಂದಿಗೆ ₹.5 ಅಂಚೆ ಚೀಟಿ (Postal Stamp) ವನ್ನು ಹೊಂದಿರುವ ಸ್ವ–ವಿಳಾಸದ ಲಕೋಟೆಯನ್ನು ಸಲ್ಲಿಸತಕ್ಕದ್ದು.
5. ಅರ್ಜಿಯೊಂದಿಗೆ ಅಭ್ಯರ್ಥಿಗಳು ತಮ್ಮ ಇತ್ತೀಚಿನ ಒಂದು ಭಾವಚಿತ್ರವನ್ನು ಸ್ವದೃಢೀಕರಿಸಿ ಲಗತ್ತಿಸಬೇಕು.
6. ಸಂದರ್ಶನ ಪತ್ರ ಬರೆದಿರುವ ಅಭ್ಯರ್ಥಿಗಳು ಸಂದರ್ಶನಕ್ಕೆ ಅರ್ಹರಲ್ಲವೆಂದು ಭಾವಿಸಿಕೊಳ್ಳತಕ್ಕದ್ದು.
7. ಆಯ್ಕೆಯ ಸಂಬಂಧವಾಗಿ ಸಂದರ್ಶನಕ್ಕೆ ಅನರ್ಹರಾದ ಅಭ್ಯರ್ಥಿಗಳು ಈ ಕಛೇರಿಯೊಂದಿಗೆ ಯಾವುದೇ ಪತ್ರ ವ್ಯವಹಾರವನ್ನು ನಡೆಸಲು ಆಸ್ಪದವಿರುವುದಿಲ್ಲ.

**ಬಿ.ಎ. ಪಾಟೀಲ್,**
ಪ್ರಧಾನ ಜಿಲ್ಲಾ ಮತ್ತು ಸತ್ರ ನ್ಯಾಯಾಧೀಶರು,
ಚಿಕ್ಕಮಗಳೂರು.

**ಅರ್ಜಿ ನಮೂನೆ**

ಪ್ರಧಾನ ಜಿಲ್ಲಾ ಮತ್ತು ಸತ್ರ ನ್ಯಾಯಾಧೀಶರು,
ಚಿಕ್ಕಮಗಳೂರು ಜಿಲ್ಲೆ,
ಚಿಕ್ಕಮಗಳೂರು – ಇವರಿಗೆ:

| ಸ್ವದೃಢೀಕರಿಸಿದ ಪಾಸ್‌ಪೋರ್ಟ್ ಅಳತೆಯ ಭಾವಚಿತ್ರವನ್ನು ಅಂಟಿಸಬೇಕು. |
|---|

ಮಾನ್ಯರೇ,

ಪ್ರಧಾನ ಜಿಲ್ಲಾ ಮತ್ತು ಸತ್ರ ನ್ಯಾಯಾಧೀಶರ ಅಧಿಸೂಚನೆ ಸಂಖ್ಯೆ: 01/2012 ದಿನಾಂಕ: 14–06–2012ರ ಪ್ರಕಾರ ನಾನು ಕೆಳಕಂಡ ಮಾಹಿತಿಗಳೊಂದಿಗೆ ಶೀಘ್ರಲಿಪಿಗಾರರು / ಬೆರಳಚ್ಚುಗಾರರ ಹುದ್ದೆಗೆ ಈ ಮೂಲಕ ನನ್ನ ವಿವರಗಳೊಂದಿಗೆ ಅರ್ಜಿ ಸಲ್ಲಿಸುತ್ತಿದ್ದೇನೆ.

| | | |
|---|---|---|
| 01 | ಅಭ್ಯರ್ಥಿಯ ಹೆಸರು<br>(ದಪ್ಪ ಅಕ್ಷರಗಳಲ್ಲಿ) | |
| 02 | ತಂದೆ / ಗಂಡನ ಹೆಸರು | |
| 03 | ತಾಯಿಯ ಹೆಸರು | |
| 04 | ಜನ್ಮ ದಿನಾಂಕ | |

| | | | | |
|---|---|---|---|---|
| 05 | ವಯಸ್ಸು<br>(ಅರ್ಜಿಯನ್ನು ಸ್ವೀಕರಿಸಲು ನಿಗದಿಪಡಿಸಿರುವ ಕೊನೆಯ ದಿನಾಂಕದಂದು ಅಭ್ಯರ್ಥಿಯ ವಯಸ್ಸು) | ವರ್ಷಗಳು | ತಿಂಗಳುಗಳು | ದಿನಗಳು |
| | | | | |

| | | |
|---|---|---|
| 06 | ಅಭ್ಯರ್ಥಿಯ ಖಾಯಂ ವಿಳಾಸ ಮತ್ತು ದೂರವಾಣಿ ಸಂಖ್ಯೆ | |
| 07 | ಲಿಂಗ | ಪುರುಷ / ಮಹಿಳೆ |
| 08 | ರಾಷ್ಟ್ರೀಯತೆ ಮತ್ತು ಧರ್ಮ | |
| 09 | ಜಾತಿ / ಉಪಜಾತಿ | |
| 10 | ವಿವಾಹಿತರಾದಲ್ಲಿ ಒಬ್ಬರಿಗಿಂತ ಹೆಚ್ಚು ಜೀವಂತ ಗಂಡ ಅಥವಾ ಹೆಂಡತಿ ಇದ್ದಾರೆಯೇ? | |
| 11 | ನೀವು ಯಾವುದಾದರೂ ಕ್ರಿಮಿನಲ್ ಮೊಕದ್ದಮೆಯಲ್ಲಿ ಭಾಗಿಯಾಗಿದ್ದೀರ? | |
| 12 | ನೀವು ಸರ್ಕಾರಿ ಸೇವೆಯಿಂದ ಅಥವಾ ಇನ್ನಾವುದಾದರೂ ಸೇವೆಯಿಂದ ವಜಾ ಆಗಿದ್ದೀರ ಅಥವಾ ತೆಗೆದುಹಾಕಲ್ಪಟ್ಟಿದ್ದೀರ? | |

| | | | | | |
|---|---|---|---|---|---|
| 13 | ಕೋರುವ ಮೀಸಲಾತಿಗಳು<br>(ಕೋರುವ ಮೀಸಲಾತಿಯನ್ನು ➡ಚಿಹ್ನೆ ಹಾಕುವುದರ ಮೂಲಕ ಗುರುತಿಸಿ ಪ್ರಮಾಣಪತ್ರದ ಸ್ವಯಂ ದೃಢೀಕೃತ ನಕಲನ್ನು ಲಗತ್ತಿಸಬೇಕು) | ಸಾಮಾನ್ಯ | ಪ.ಜಾತಿ | ಪ.ಪಂಗಡ | ಪ್ರವರ್ಗ–1 |
| | | | | | |
| | | 2–ಎ | 2–ಬಿ | 3–ಎ | 3–ಬಿ |
| | | | | | |

| | | | | | | |
|---|---|---|---|---|---|---|
| 14 | ನೀವು ಈ ಯಾವುದಾದರೂ ಮೀಸಲಾತಿ ಅಡಿಯಲ್ಲಿ ಬರುತ್ತೀರ?<br>(ಸೇರುವ ಮೀಸಲಾತಿಯನ್ನು ➡ಚಿಹ್ನೆ ಹಾಕುವುದರ ಮೂಲಕ ಗುರುತಿಸಿ ಪ್ರಮಾಣಪತ್ರದ ಸ್ವಯಂ ದೃಢೀಕೃತ ನಕಲನ್ನು ಲಗತ್ತಿಸಬೇಕು) | ಗ್ರಾಮೀಣ | ಕ.ಮಾ.ಅ. | ಮಾ.ಸೈ. | ಅಂ.ಅ. | ಯೋ.ನಿ.ಅ. |
| | | | | | | |

| | | | | | |
|---|---|---|---|---|---|
| 15 | ಶೈಕ್ಷಣಿಕ ವಿದ್ಯಾರ್ಹತೆ<br>(ಅನ್ವಯಿಸುವ ವಿದ್ಯಾರ್ಹತೆಯ ಅಂಕಣಗಳನ್ನು ಮಾತ್ರ ಭರ್ತಿ ಮಾಡುವುದು)<br>(ಸ್ವಯಂ ದೃಢೀಕೃತ ಪ್ರಮಾಣ ಪತ್ರಗಳನ್ನು ಸಲ್ಲಿಸತಕ್ಕದ್ದು) | ಉತ್ತೀರ್ಣ ಹೊಂದಿದ ವರ್ಷ | ಗರಿಷ್ಠ ಅಂಕಗಳು | ಗಳಿಸಿದ ಅಂಕಗಳು | ಶೇಕಡಾ ವಾರು ಅಂಕಗಳು |
| | ಎಸ್‌ಎಸ್‌ಎಲ್‌ಸಿ | | | | |
| | ಕನ್ನಡ ಬೆರಳಚ್ಚು (ಹಿರಿಯ ಶ್ರೇಣಿ) | | | | |
| | ಆಂಗ್ಲ ಬೆರಳಚ್ಚು (ಹಿರಿಯ ಶ್ರೇಣಿ) | | | | |
| | ಕನ್ನಡ ಶೀಘ್ರಲಿಪಿ (ಹಿರಿಯ ಶ್ರೇಣಿ) | | | | |
| | ಆಂಗ್ಲ ಶೀಘ್ರಲಿಪಿ (ಹಿರಿಯ ಶ್ರೇಣಿ) | | | | |
| | ಕಂಪ್ಯೂಟರ್ ಶಿಕ್ಷಣದ ಬಗ್ಗೆ | | | | |

**ಸೂಚನೆಃ**– ಅಭ್ಯರ್ಥಿಗಳು ಎಲ್ಲಾ ಕಾಲಂಗಳನ್ನು ಖಡ್ಡಾಯವಾಗಿ ಭರ್ತಿ ಮಾಡತಕ್ಕದ್ದು.

**: ಘೋಷಣೆ :**

ಈ ಮೇಲೆ ನಮೂದಿಸಿರುವ ಮಾಹಿತಿ ಮತ್ತು ವಿವರಗಳು ಸತ್ಯವಾಗಿದ್ದು ಒಂದು ವೇಳೆ ಅವು ಅಸತ್ಯವೆಂದು ಕಂಡು ಬಂದಲ್ಲಿ ತಾವು ತೆಗೆದುಕೊಳ್ಳುವ ತೀರ್ಮಾನಗಳಿಗೆ ಬದ್ಧನಾಗಿರುತ್ತೇನೆ / ಬದ್ಧಳಾಗಿರುತ್ತೇನೆ. ನಾನು ಆಯ್ಕೆಗೊಂಡ ಪಕ್ಷದಲ್ಲಿ ಚಿಕ್ಕಮಗಳೂರು ಜಿಲ್ಲೆಯ ಯಾವುದೇ ನ್ಯಾಯಾಲಯಗಳಲ್ಲಿ ಕರ್ತವ್ಯ ನಿರ್ವಹಿಸಲು ಸಿದ್ಧನಿರುತ್ತೇನೆ/ಸಿದ್ಧಳಿರುತ್ತೇನೆ.

ಸ್ಥಳಃ

ದಿನಾಂಕಃ ಅಭ್ಯರ್ಥಿಯ ಸಹಿ.

**ಪಿ.ಆರ್. 103**

## ಜಿಲ್ಲಾಧಿಕಾರಿಗಳು ಹಾಗೂ ಅಧ್ಯಕ್ಷರು, ಗ್ರಾಮಲೆಕ್ಕಿಗರ ನೇರನೇಮಕಾತಿ ಆಯ್ಕೆ ಪ್ರಾಧಿಕಾರ, ಕೋಲಾರ ಜಿಲ್ಲೆ, ಕೋಲಾರ

### ಅಧಿಸೂಚನೆ

**ಅಧಿಸೂಚನೆ ನಂ. ಸಿಬ್ಬಂದಿ(2) ಸಿಆರ್:15/2012–13, ದಿನಾಂಕ 29/06/2012**

**ವಿಷಯ :** ಕೋಲಾರ ಜಿಲ್ಲಾ ಕಂದಾಯ ಇಲಾಖೆಯಲ್ಲಿ ಖಾಲಿ ಇರುವ ಗ್ರಾಮಲೆಕ್ಕಿಗರ ಹುದ್ದೆಗಳನ್ನು ನೇರನೇಮಕಾತಿ ಮೂಲಕ ಭರ್ತಿ ಮಾಡುವ ಬಗ್ಗೆ

**ಉಲ್ಲೇಖ :** ಸರ್ಕಾರದ ಅಧಿಸೂಚನೆ ನಂ. ಆರ್‌ಡಿ 299 ಬಿಎಸ್‌ಸಿ 2006 ದಿನಾಂಕ 3/2/2009

2. ಈ ಪ್ರಾಧಿಕಾರದ ಅಧಿಸೂಚನೆ ಸಂಖ್ಯೆ ಸಿಬ್ಬಂದಿ(2) ಸಿಆರ್. 88/2008–09 ದಿನಾಂಕ 26/9/2009
3. ನೇಮಕಾತಿ ಅಧಿಸೂಚನೆ ನಂ. ಸಿಬ್ಬಂದಿ(2) ಸಿಆರ್. 88 /2008–09 ದಿನಾಂಕ 31/12/2009
4. ಸರ್ಕಾರದ ಪತ್ರ ನಂ. ಕಂಇ 4 ಬಿಎಸ್‌ಸಿ 2011 ದಿನಾಂಕ 25/2/2011
5. ಸರ್ಕಾರದ ಆದೇಶ ಸಂಖ್ಯೆ ಕಂಇ 33 ಡಿಎಸ್‌ಪಿ 2012 ದಿನಾಂಕ 5/6/2012

ಕೋಲಾರ ಜಿಲ್ಲಾ ಘಟಕ, ಕಂದಾಯ ಇಲಾಖೆಯಲ್ಲಿ ಖಾಲಿ ಇರುವ ಗ್ರಾಮಲೆಕ್ಕಿಗರ ಹುದ್ದೆಗಳನ್ನು ನೇರನೇಮಕಾತಿ ಮೂಲಕ ಭರ್ತಿ ಮಾಡಲು ಉಲ್ಲೇಖ (4) ರಂತೆ ಸರ್ಕಾರ ಅನುಮತಿ ನೀಡಿರುತ್ತದೆ. ಇಲಾಖೆಯಲ್ಲಿ ಗ್ರಾಮಲೆಕ್ಕಿಗರ ವಯೋನಿವೃತ್ತಿ, ಮುಂಬಡ್ತಿ, ವರ್ಗಾವಣೆ ಹಾಗೂ ಇನ್ನಿತರೆ ಕಾರಣಗಳಿಂದಾಗಿ 41 ಹುದ್ದೆಗಳು ತೆರವಾಗಿವೆ. ಹೊಸದಾಗಿ ನಾಡಕಛೇರಿಗಳ ರಚನೆಗೆ ಸಂಬಂಧಿಸಿದಂತೆ ಉಲ್ಲೇಖ (5) ರನ್ವಯ ಈ ಜಿಲ್ಲೆಗೆ 12 ಗ್ರಾಮಲೆಕ್ಕಿಗರ ಹುದ್ದೆಗಳು ಮಂಜೂರಾಗಿರುತ್ತದೆ. ಆದುದರಿಂದ ಒಟ್ಟು 53 ಗ್ರಾಮಲೆಕ್ಕಾಧಿಕಾರಿಗಳ ಹುದ್ದೆಗಳನ್ನು ಕರ್ನಾಟಕ ಸಾಮಾನ್ಯ ಸೇವೆಗಳು (ರೆವಿನ್ಯೂ ಸಬಾರ್ಡಿನೇಟ್ ಬ್ರಾಂಚ್) (ಕೇಡರ್ ಅಂಡ್ ರಿಕ್ರ್ಯೂಟ್‌ಮೆಂಟ್) (ತಿದ್ದುಪಡಿ) ನಿಯಮಗಳು 2008 ರನ್ವಯ ನೇರನೇಮಕಾತಿ ಮೂಲಕ ಭರ್ತಿಮಾಡಲು ಸರ್ಕಾರದ ಪತ್ರ ನಂ. ಕಂಇ 4 ಬಿಎಸ್‌ಸಿ 2011 ದಿನಾಂಕ 25/2/2011 ರಲ್ಲಿ ಅನುಮೋದನೆ ನೀಡಿದೆ. ಅದರಂತೆ 41 ಪಿಯುಸಿ ವಿದ್ಯಾರ್ಹತೆ ಹಾಗೂ 12 ಪಿಯುಸಿ ಮತ್ತು ಕಂಪ್ಯೂಟರ್ ಜ್ಞಾನವಿರುವಂತೆ ಒಟ್ಟು 53 ಗ್ರಾಮಲೆಕ್ಕಾಧಿಕಾರಿಗಳ ಹುದ್ದೆಗಳನ್ನು ನೇರನೇಮಕಾತಿಯಿಂದ ಭರ್ತಿ ಮಾಡಲು ಅರ್ಹ ಅಭ್ಯರ್ಥಿಗಳಿಂದ ಅರ್ಜಿಯನ್ನು ಅಹ್ವಾನಿಸಲಾಗಿದೆ.

ಅರ್ಹ ಅಭ್ಯರ್ಥಿಗಳು ನಿಗಧಿತ ನಮೂನೆಯಲ್ಲಿ ಅನ್‌ಲೈನ್ ಮೂಲಕ ಎಲ್ಲಾ ವಿವರಗಳೊಂದಿಗೆ ಭರ್ತಿ ಮಾಡಿದ ಅರ್ಜಿಗಳನ್ನು ಸಲ್ಲಿಸಲು **ಕೊನೆಯ ದಿನಾಂಕ 08/08/2012.**

ಹುದ್ದೆಗಳ ಸಂಖ್ಯೆಯನ್ನು ಕಡಿಮೆ ಅಥವಾ ಹೆಚ್ಚು ಮಾಡುವುದಕ್ಕೆ ಜಿಲ್ಲಾಧಿಕಾರಿಗಳಿಗೆ ಮಾತ್ರ ಅಧಿಕಾರವಿರುತ್ತದೆ.

**ಗ್ರಾಮಲೆಕ್ಕಿಗರ ಹುದ್ದೆಗಳ ವಿವರ**

| ಕ್ರ.ಸಂ. | ಹುದ್ದೆಯ ಹೆಸರು | ಒಟ್ಟು ಹುದ್ದೆ | ವಿದ್ಯಾರ್ಹತೆ | ವೇತನಶ್ರೇಣಿ |
|---|---|---|---|---|
| 1 | ಗ್ರಾಮಲೆಕ್ಕಾಧಿಕಾರಿ | 41 | ಪಿಯುಸಿ ಅಥವಾ (ಸಿಬಿಎಸ್‌ಇ/ಐಸಿಎಸ್‌ಇ) 12ನೇ ತರಗತಿ ಪರೀಕ್ಷೆಯಲ್ಲಿ ಉತ್ತೀರ್ಣರಾಗಿರಬೇಕು | 11600–200–12000–250–13000–300–14200–350–15600–400–17200–450–19000–500–21000 |
| 2 | ಗ್ರಾಮಲೆಕ್ಕಾಧಿಕಾರಿ (ನಾಡಕಛೇರಿಗಳಿಗೆ) | 12 | ಪಿಯುಸಿ ಅಥವಾ (ಸಿಬಿಎಸ್‌ಇ/ಐಸಿಎಸ್‌ಇ) 12ನೇ ತರಗತಿ ಪರೀಕ್ಷೆಯಲ್ಲಿ ಉತ್ತೀರ್ಣರಾಗಿರಬೇಕು ಹಾಗೂ Computer Fundamentals MS WINDOWS, MS WORD, MS EXCEL, MS-ACCESS, POWER POINT & INTERNET ಬಗ್ಗೆ ಅಂಗೀಕೃತ ಸಂಸ್ಥೆಯಿಂದ ಪ್ರಮಾಣಪತ್ರಗಳನ್ನು ಪಡೆದಿರಬೇಕು | |

**ಷರಾ :** Must have passed Pre-University Examiniation or 12th standard examination conducted by Central Board of Secondary Education or ICSE (Notification No. RD 299 BSC 2006 dt: 24/7/09)

ಮೀಸಲಾತಿ ವರ್ಗೀಕರಣ

2012–13ನೇ ಸಾಲಿನಲ್ಲಿ ಖಾಲಿ ಇರುವ ಗ್ರಾಮಲೆಕ್ಕಿಗರ ಹುದ್ದೆಗಳ ವರ್ಗೀಕರಣ

| ಕ್ರ.ಸಂ | ಮೀಸಲಾತಿ | ಸಾಮಾನ್ಯ | ಮಹಿಳೆ | ಗ್ರಾಮೀಣ | ಅಂಗವಿಕಲ | ಮಾಜಿಸೈನಿಕ | ಕನ್ನಡ ಮಾಧ್ಯಮ | ಯೋಜನಾ ನಿರಾಶ್ರಿತರು | ಒಟ್ಟು |
|---|---|---|---|---|---|---|---|---|---|
| 1 | ಪರಿಶಿಷ್ಟ ಜಾತಿ | 1 | 2 | 2 | 0 | 1 | 0 | 0 | **6** |
| 2 | ಪರಿಶಿಷ್ಟ ಪಂಗಡ | – | – | 1 | – | – | – | – | **1** |
| 3 | ಪ್ರವರ್ಗ 1 | – | – | 1 | 1 | – | – | – | **2** |
| 4 | ಪ್ರವರ್ಗ 2(ಎ) | 1 | 2 | 2 | – | 1 | – | – | **6** |
| 5 | ಪ್ರವರ್ಗ 2(ಬಿ) | – | – | 1 | 1 | – | – | – | **2** |
| 6 | ಪ್ರವರ್ಗ 3(ಎ) | – | – | 1 | – | – | – | – | **1** |
| 7 | ಪ್ರವರ್ಗ 3(ಬಿ) | – | – | 1 | 1 | – | – | – | **2** |
| 8 | ಸಾಮಾನ್ಯ | 4 | 6 | 5 | 2 | 2 | 1 | 1 | **21** |
| **ಒಟ್ಟು** | | **6** | **10** | **14** | **5** | **4** | **1** | **1** | **41** |

2012–13ನೇ ಸಾಲಿನಲ್ಲಿ ಹೊಸದಾಗಿ ರಚನೆಗೊಳ್ಳುವ ನಾಡಕಛೇರಿಗಳಿಗೆ ಕಂಪ್ಯೂಟರ್‌ಜ್ಞಾನ ಹೊಂದಿರುವ ಗ್ರಾಮಲೆಕ್ಕಿಗರ ಹುದ್ದೆಗಳ ವರ್ಗೀಕರಣ

| ಕ್ರ.ಸಂ | ಮೀಸಲಾತಿ | ಸಾಮಾನ್ಯ | ಮಹಿಳೆ | ಗ್ರಾಮೀಣ | ಅಂಗವಿಕಲ | ಮಾಜಿಸೈನಿಕ | ಕನ್ನಡ ಮಾಧ್ಯಮ | ಯೋಜನಾ ನಿರಾಶ್ರಿತರು | ಒಟ್ಟು |
|---|---|---|---|---|---|---|---|---|---|
| 1 | ಪರಿಶಿಷ್ಟ ಜಾತಿ | – | 1 | – | – | – | 1 | – | **2** |
| 2 | ಪರಿಶಿಷ್ಟ ಪಂಗಡ | – | – | – | – | – | – | – | – |
| 3 | ಪ್ರವರ್ಗ 1 | – | – | – | – | – | – | – | – |
| 4 | ಪ್ರವರ್ಗ 2(ಎ) | – | 1 | – | – | – | 1 | – | **2** |
| 5 | ಪ್ರವರ್ಗ 2(ಬಿ) | – | – | – | – | – | – | – | – |
| 6 | ಪ್ರವರ್ಗ 3(ಎ) | – | – | – | 1 | – | – | – | **1** |
| 7 | ಪ್ರವರ್ಗ 3(ಬಿ) | – | 1 | – | – | – | – | – | **1** |
| 8 | ಸಾಮಾನ್ಯ | 1 | 2 | 2 | – | 1 | – | – | **6** |
| **ಒಟ್ಟು** | | **1** | **5** | **2** | **1** | **1** | **2** | – | **12** |

**ಅಭ್ಯರ್ಥಿಗಳಿಗೆ ಸೂಚನೆ ಮತ್ತು ಷರತ್ತುಗಳು:**

1. **ಅರ್ಜಿ ನಮೂನೆ:** ಅರ್ಹ ಅಭ್ಯರ್ಥಿಗಳು ಅರ್ಜಿಗಳನ್ನು ಅನ್‌ಲೈನ್ (online) ಮುಖಾಂತರ ಮಾತ್ರ ಸಲ್ಲಿಸತಕ್ಕದ್ದಾಗಿದೆ.

   ಅರ್ಜಿಗಳನ್ನು ಖುದ್ದಾಗಿಯಾಗಲೀ ಅಥವಾ ಅಂಚೆ ಮೂಲಕ ಆಗಲೀ ಸಲ್ಲಿಸಲು ಅವಕಾಶವಿರುವುದಿಲ್ಲ. ಅಭ್ಯರ್ಥಿಯ ಕಛೇರಿಯ ಅಧಿಕೃತ ವೆಬ್‌ಸೈಟ್‌ಗಳಾದ http://recruitment.kar.nic.in ನ ಅನ್‌ಲೈನ್ ಮುಖಾಂತರ ಗ್ರಾಮಲೆಕ್ಕಿಗರ ನೇರನೇಮಕಾತಿ ಅರ್ಜಿ ತುಂಬುವುದು ರ ಮೇಲೆ ಕ್ಲಿಕ್ ಮಾಡಿದಾಗ ತೆರದ ಕಂಪ್ಯೂಟರ್ ಪರದೆಯ ಮೇಲೆ ಅರ್ಜಿಯನ್ನು ತುಂಬಬೇಕು. ಅರ್ಜಿಯನ್ನು ಭರ್ತಿ ಮಾಡಿದ ನಂತರ ಅಭ್ಯರ್ಥಿಯು submit button ನ್ನು ಒತ್ತಿದರೆ ಅರ್ಜಿ ಸಂಖ್ಯೆ (reference number) ಸೃಷ್ಟಿಯಾಗುತ್ತದೆ. ಅನ್‌ಲೈನ್ ಅರ್ಜಿಯನ್ನು ಭರ್ತಿ ಮಾಡಿದ ನಂತರ ಅಭ್ಯರ್ಥಿಗಳು ಸ್ವೀಕೃತಿ ಪತ್ರ (acknowledgement slip) ಮತ್ತು ಚಲನ್‌ನ ದ್ವಿಪ್ರತಿಗಳನ್ನು ತೆಗೆದುಕೊಳ್ಳತಕ್ಕದ್ದು, ಈ ಚಲನ್‌ನ್ನು ಅರ್ಜಿ ಶುಲ್ಕದೊಂದಿಗೆ **ಸ್ಟೇಟ್ ಬ್ಯಾಂಕ್ ಆಫ್ ಮೈಸೂರ್‌ನ** ಯಾವುದೇ ಶಾಖೆಯಲ್ಲಿ ಪಾವತಿಸಬಹುದು. ಪಾವತಿಸುವಾಗ ಚಲನ್‌ನಲ್ಲಿ ಅರ್ಜಿಯ ಸಂಖ್ಯೆ (reference number) ಮತ್ತು ಅಭ್ಯರ್ಥಿಯ ಹೆಸರು ಸರಿಯಾಗಿ ನಮೂದಾಗಿದೆಯೇ ಎಂದು ಅಭ್ಯರ್ಥಿಯು ಪರಿಶೀಲಿಸುವುದು. ಅಭ್ಯರ್ಥಿಗಳು ಸ್ವೀಕೃತಿ ಪತ್ರವನ್ನು ಮತ್ತು ಚಲನ್‌ಪಾವತಿಯ ಒಂದು ಪ್ರತಿಯನ್ನು ಕಡ್ಡಾಯವಾಗಿ ತಮ್ಮ ಬಳಿ ಇರಿಸಿಕೊಳ್ಳತಕ್ಕದ್ದು. ಅರ್ಜಿ ಶುಲ್ಕದ ಜೊತೆಗೆ ಬ್ಯಾಂಕ್ ಸರ್ವೀಸ್ ಚಾರ್ಜ್‌ನ್ನು ಸಹಾ ಅಭ್ಯರ್ಥಿಗಳು ಬ್ಯಾಂಕ್‌ಗೆ ಪಾವತಿಸತಕ್ಕದ್ದು. ಈ ದಾಖಲೆಗಳನ್ನು ಪರಿಶೀಲನೆಗೆ ನಿಗದಿಪಡಿಸಿದ ದಿನಾಂಕದಂದು ಹಾಜರುಪಡಿಸತಕ್ಕದ್ದು. ಅನ್‌ಲೈನ್ ಮೂಲಕ ಅರ್ಜಿಗಳನ್ನು ಸಲ್ಲಿಸಲು ಕೊನೆಯ ದಿನಾಂಕ 8/8/2012 ಆಗಿರುತ್ತದೆ. ಬ್ಯಾಂಕಿನಲ್ಲಿ ನಿಗದಿತ ಅರ್ಜಿ ಶುಲ್ಕ ಪಾವತಿಸಲು ಕೊನೆಯ ದಿನಾಂಕ 9/8/2012 ಆಗಿರುತ್ತೆ.

ಆಯ್ಕೆ ಪ್ರಕ್ರಿಯೆ ಪೂರ್ಣಗೊಂಡ ನಂತರ, ಆಯ್ಕೆಯಾದ ಅಭ್ಯರ್ಥಿಗಳ ಮೂಲ ದಾಖಲಾತಿಗಳ ಪರಿಶೀಲನೆಗಾಗಿ ದಿನಾಂಕ ನಿಗದಿಪಡಿಸಲಾಗುವುದು. ಅರ್ಜಿಯಲ್ಲಿ ಕಾಣಿಸಲಾದ ಎಲ್ಲಾ ನಿಗದಿತ ದಾಖಲೆಗಳ ಮೂಲಪ್ರತಿಗಳನ್ನು ಕಡ್ಡಾಯವಾಗಿ ಹಾಜರುಪಡಿಸತಕ್ಕದ್ದು. ಇಲ್ಲದಿದ್ದಲ್ಲಿ ಅಂತಹವರುಗಳ ಅರ್ಜಿಗಳನ್ನು ತಿರಸ್ಕರಿಸಲಾಗುವುದು. ಅಭ್ಯರ್ಥಿಗಳು ಮೂಲ ದಾಖಲಾತಿಗಳನ್ನು ಹಾಜರುಪಡಿಸುವ ಸಂದರ್ಭದಲ್ಲಿ ಆಯ್ಕೆ ಪಟ್ಟಿಯ ಪ್ರತಿಯನ್ನು ಮೇಲ್ಕಂಡ ವೆಬ್‌ಸೈಟ್‌ನಿಂದ ಪಡೆದು ಹಾಜರುಪಡಿಸತಕ್ಕದ್ದು.

ಅಭ್ಯರ್ಥಿಯ ಜನ್ಮ ದಿನಾಂಕವನ್ನು ಎಸ್.ಎಸ್.ಎಲ್.ಸಿ. ಅಥವಾ ತತ್ಸಮಾನ ವಿದ್ಯಾರ್ಹತೆಯ ಪ್ರಮಾಣಪತ್ರ, ವರ್ಗಾವಣೆ ಪ್ರಮಾಣಪತ್ರ (ಟಿ.ಸಿ) ಕ್ಯುಮುಲೇಟಿವ್, ರೆಕಾರ್ಡ್‌ನಲ್ಲಿ ನಮೂದಿಸಿರುವಂತೆ ಪರಿಗಣಿಸಲಾಗುವುದು. ಇತರೆ ಯಾವುದೇ ದಾಖಲೆಗಳನ್ನು ಪರಿಗಣಿಸಲಾಗುವುದಿಲ್ಲ.

2. **ವಯೋಮಿತಿ:** ಅರ್ಜಿಗಳನ್ನು ಸ್ವೀಕರಿಸಲು ನಿಗದಿಪಡಿಸಿದ ಕೊನೆಯ ದಿನಾಂಕದಂದು ಅಭ್ಯರ್ಥಿಯು

**ಅ) ಕನಿಷ್ಠ** 18 ವರ್ಷ ವಯಸ್ಸನ್ನು ಪೂರೈಸಿರತಕ್ಕದ್ದು.

**ಆ) ಗರಿಷ್ಠ ವಯೋಮಿತಿ ಈ ಕೆಳಕಂಡಂತಿರತಕ್ಕದ್ದು.**

| | |
|---|---|
| ಸಾಮಾನ್ಯ ವರ್ಗ | 35 ವರ್ಷ |
| 2ಎ, 2ಬಿ, 3ಎ, 3ಬಿ | 38 ವರ್ಷ |
| ಪಜಾ/ ಪಪಂ/ ಪ್ರ–1 | 40 ವರ್ಷ |
| ವಿಧವೆಯರು / ಅಂಗವಿಕಲ | ಚಾಲ್ತಿಯಲ್ಲಿ ನಿಗದಿಪಡಿಸಿರುವ ವಯೋಮಿತಿಗೆ 10 ವರ್ಷ ಹೆಚ್ಚಿಗೆ ಸೇರಿಸಿಕೊಳ್ಳಲಾಗುವುದು.. |

**ಈ ಕೆಳಗಿನ ಸಂದರ್ಭಗಳಲ್ಲಿ ನೇಮಕಾತಿಯ ಗರಿಷ್ಠ ವಯೋಮಿತಿಯನ್ನು ಕೆಳಗೆ ತಿಳಿಸಿದಷ್ಟು ಮಟ್ಟಿಗೆ ಹೆಚ್ಚಿಸಲಾಗುವುದು:**

- **ಮಾಜಿ ಸೈನಿಕರು:** ಅಭ್ಯರ್ಥಿಯು ಮಾಜಿ ಸೈಜನಿಕನಾಗಿದ್ದಲ್ಲಿ ಸಶಸ್ತ್ರದಳದಲ್ಲಿ ಎಷ್ಟು ವರ್ಷ ಸೇವೆ ಸಲ್ಲಿಸಿರುವನೋ ಆ ವರ್ಷಗಳಿಗೆ ಮೂರು ವರ್ಷಗಳನ್ನು ಸೇರಿಸಿದರೆ ಎಷ್ಟು ವರ್ಷಗಳಾಗುವುದೋ ಅಷ್ಟು ವರ್ಷಗಳು.

**ವಿವರಣೆ:** (ಎ) ಮಾಜಿ ಸೈನಿಕ ಎಂದರೆ ಸಶಸ್ತ್ರದಳಗಳಾದ ನಿಯಮಿತ ಭೂದಳ, ನೌಕಾದಳ ಮ್ತು ವಾಯುದಳದಲ್ಲಿ ಯಾವುದೇ ಶ್ರೇಣಿಯಲ್ಲಿ (ಯೋಧ ಮತ್ತು ಅಯೋಧನಾಗಿ) ಸೇವೆ ಸಲ್ಲಿಸಿದ ವ್ಯಕ್ತಿ ಅಂದರೆ ಡಿಫೆನ್ಸ್ ಸೆಕ್ಯೂರಿಟಿ ಕೋರ್, ಜನರಲ್ ರಿಸರ್ವ್ ಇಂಜಿನಿಯರಿಂಗ್ ಜಪೋಸ, ಲೋಕಸಹಾಯಕ ಸೇನಾ ಮತ್ತು ಪ್ಯಾರಾ ಮಿಲಿಟರಿ ದಳದಲ್ಲಿ ಸೇವೆ ಸಲ್ಲಿಸಿದ ವ್ಯಕ್ತಿ ಸೇರ್ಪಡೆಯಾಗುವುದಿಲ್ಲ ಮತ್ತು ಕೇಂದ್ರ ಸಶಸ್ತ್ರದಳಗಳಲ್ಲಿ ಸೇವೆ ಸಲ್ಲಿಸುವಾಗ ಕೊಲ್ಲಲ್ಪಟ್ಟ ಅಥವಾ ಶಾಶ್ವತವಾಗಿ ದೈಹಿಕ ವಿಕಲತೆ ಹೊಂದಿದ ವ್ಯಕ್ತಿಗಳ ಕುಟುಂಬದವರು (ಸಂದರ್ಭಾನುಸಾರ ಹೆಂಡತಿ ಅಥವಾ ಗಂಡ ಮತ್ತು ಮಕ್ಕಳು ಮತ್ತು ಮಲ ಮಕ್ಕಳು) ಮಾಜಿ ಸೈನಿಕ ಮೀಸಲಾತಿಗೆ ಅರ್ಹರಾಗಿರುತ್ತಾರೆ. ಆದರೆ ಅಂತಹವರುಗಳಿಗೆ ವಯೋಮಿತಿ ಸಡಿಲಿಕೆಯನ್ನು ನೀಡಲಾಗುವುದಿಲ್ಲ.

ಅ) ಅಂತಹ ಸೇನೆಯಿಂದ ನಿವೃತ್ತಿ ಹೊಂದಿದ ನಂತರ ನಿವೃತ್ತಿ ವೇತನ ಪಡೆಯುತ್ತಿರುವ ಅಥವಾ

ಆ) ವೈದ್ಯಕೀಯ ಕಾರಣಗಳಿಂದ ಮಿಲಿಟರಿ ಸೇವೆಗಳಿಂದ ಬಿಡುಗಡೆಯಾದ ಅಥವಾ ವ್ಯಕ್ತಿಯ ಹಿಡಿತಕ್ಕೂ ಮೀರಿದ ಪರಿಸ್ಥಿತಿಗಳಿಂದ ಮತ್ತು ವೈದ್ಯಕೀಯ ಮತ್ತು ಸಾಮರ್ಥ್ಯದ ಪಿಂಚಣಿ ಪಡೆದು ಸೇವೆಯಲ್ಲಿ ಬಿಡುಗಡೆಯಾದವನು ಅಥವಾ

ಇ) ಸ್ವಂತ ಕೋರಿಕೆ ಹೊರತುಪಡಿಸಿ ಸಿಬ್ಬಂದಿ ಕಡಿತದ ಪರಿಣಾಮದಿಂದ ಅಂತಹ ಸೇನೆಯಿಂದ ಬಿಡುಗಡೆ ಹೊಂದಿದ ವ್ಯಕ್ತಿ ಅಥವಾ

ಈ) ತನ್ನ ಸ್ವಂತ ಕೋರಿಕೆ ಮೇರೆಗೆ ಅಥವಾ ದುರ್ನಡತೆ ಅಥವಾ ಅಸಾಮರ್ಥ್ಯದ ಕಾರಣದಿಂದಾಗಿ ತೆಗೆದುಹಾಕಿರುವ ಅಥವಾ ಕರ್ತವ್ಯದಿಂದ ವಜಾ ಮಾಡಿದ ವ್ಯಕ್ತಿಗಳನ್ನು ಹೊರತುಪಡಿಸಿ, ನಿರ್ದಿಷ್ಟ ಅವಧಿಯನ್ನು ಪೂರೈಸಿದ ತರುವಾಯ ಬಿಡುಗಡೆ ಹೊಂದಿದ ವ್ಯಕ್ತಿ ಮತ್ತು ಗ್ರಾಚುಟಿ ಪಡೆಯುತ್ತಿರುವ ವ್ಯಕ್ತಿ ಮತ್ತು ಪ್ರಾಂತೀಯ ಸೇವೆಯ ಈ ಕೆಳಗೆ ಹೆಸರಿಸಿದ ವರ್ಗದ ಸಿಬ್ಬಂದಿಯವರು.

1. ನಿರಂತರ ಸೇವೆ ಸಲ್ಲಿಸಿ ನಿವೃತ್ತಿ ಹೊಂದಿದ ಪಿಂಚಣಿದಾರರು
2. ಮಿಲಿಟರಿ ಸೇವೆಯಿಂದಾಗಿ ಉಂಟಾದ ದೈಹಿಕ ಅಸಾಮರ್ಥ್ಯತೆ ಹೊಂದಿ ಬಿಡುಗಡೆಯಾದ ವ್ಯಕ್ತಿ
3. ಗ್ಯಾಲೆಂಟ್ರಿ ಪ್ರಶಸ್ತಿ ವಿಜೇತರು

**ವಿವರಣೆ:** ಕೇಂದ್ರ ಸಶಸ್ತ್ರದಳದ ಸೇವೆಯಲ್ಲಿ ವ್ಯಕ್ತಿಗಳು ಸೇವೆಯಿಂದ ನಿವೃತ್ತಿಹೊಂದಿದ ನಂತರ ಮಾಜಿ ಸೈನಿಕರ ವರ್ಗದಡಿ ಬರುವ ವ್ಯಕ್ತಿಗೆ ಒಪ್ಪಂದವು ಪೂರ್ಣವಾಗಲು ಒಂದು ವರ್ಷಕ್ಕೆ ಮುನ್ನ ಉದ್ಯೋಗಕ್ಕೆ ಅರ್ಜಿ ಹಾಕಿಕೊಳ್ಳಲು ಹಾಗೂ ಅವರಿಗೆ ಮಾಜಿ ಸೈನಿಕರಿಗೆ ದೊರೆಯುವ ಎಲ್ಲಾ ಸೌಲಭ್ಯಗಳನ್ನು ಹೊಂದಲು ಅನುಮತಿ ನೀಡಲಾಗಿದೆ. ಆದರೆ, ಸಮವಸ್ತ್ರವನ್ನು ತ್ಯಜಿಸಲು ಅನುಮತಿ ನೀಡುವವರೆಗೆ ರಾಜ್ಯ ನಾಗರೀಕ ಸೇವೆ ಅಥವಾ ಹುದ್ದೆಗಳಿಗೆ ನೇಮಕ ಹೊಂದುವಂತಿಲ್ಲ.

- ಅಭ್ಯರ್ಥಿಯು ನ್ಯಾಷನಲ್ ಕೆಡೆಟ್ ಕಾರ್ಪ್ಸ್‌ನಲ್ಲಿ ಪೂರ್ಣ ಕಾಲಿಕ ಪರಿವೀಕ್ಷಕನಾಗಿ ಸೇವೆ ಸಲ್ಲಿಸಿ ಬಿಡುಗಡೆಯಾಗಿರುವ ವ್ಯಕ್ತಿಯಾಗಿದ್ದರೆ ಅಂತಹ ಕ್ಯಾಡೆಟ್ ಪರಿವೀಕ್ಷಕನಾಗಿ ಸೇವೆ ಸಲ್ಲಿಸಿದಷ್ಟು ವರ್ಷಗಳು.
- ಅಭ್ಯರ್ಥಿಯು ರಾಜ್ಯಸರ್ಕಾರದಿಂದ ಪುರಸ್ಕೃತವಾದ ಗ್ರಾಮೀಣ ಔದ್ಯಮೀಕರಣ ಯೋಜನೆಯ ಮೇರೆಗೆ ನೇಮಕಗೊಂಡು ಗ್ರಾಮಸಮೂಹ ಪರಿಶೀಲಕರಾಗಿ ಈಗ ಕೆಲಸ ಮಾಡುತ್ತಿದ್ದರೆ, ಅಥವಾ ಹಿಂದೆಯಿದ್ದ ಪಕ್ಷದಲ್ಲಿ ಅಂತಹ ಗ್ರಾಮ ಸಮೂಹ ಪರಿಶೀಲಕರಾಗಿ ಸೇವೆ ಸಲ್ಲಿಸಿದಷ್ಟು ವರ್ಷಗಳು.
- ಅಭ್ಯರ್ಥಿಯು ಜೀತಕಾರ್ಮಿಕನಾಗಿದ್ದ ಪಕ್ಷದಲ್ಲಿ 10 ವರ್ಷಗಳು
- ಜೀತ ಕಾರ್ಮಿಕನಾಗಿದ್ದ ಅಭ್ಯರ್ಥಿಯು ವಯೋಮಿತಿ ಸಡಿಲಿಕೆ ಪಡೆಯಲು ಸದರಿ ಅಧಿನಿಯಮ ಅಥವಾ 1957 ರ ಕರ್ನಾಟಕ ಜೀತ ಕಾರ್ಮಿಕ ಪದ್ಧತಿ (ರದ್ದಿಯಾತಿ) ಆದೇಶದ ಮೇರೆಗೆ ಜೀತ ಸಾಲವನ್ನು ಸಂದಾಯ ಮಾಡುವ ಹೊಣೆಯಿಂದ ಬಿಡುಗಡೆಯಾಗಿದ್ದಾನೆಂದು ಪ್ರಮಾಣ ಪತ್ರವನ್ನು ಜಿಲ್ಲಾ ಮ್ಯಾಜಿಸ್ಟ್ರೇಟ್‌ರಿಂದ ಪಡೆದಿಟ್ಟು ಕೊಂಡಿರತಕ್ಕದ್ದು.
- ಅಭ್ಯರ್ಥಿಯು ಕರ್ನಾಟಕ ರಾಜ್ಯದಲ್ಲಿರುವ ಭಾರತ ಸರ್ಕಾರದ ಜನಗಣತಿ ಸಂಸ್ಥೆಯಲ್ಲಿ ಈಗ ಹುದ್ದೆಯನ್ನು ಹೊಂದಿದ್ದರೆ ಅಥವಾ ಹಿಂದೆ ಹೊಂದಿದ್ದ ಪಕ್ಷದಲ್ಲಿ ಗರಿಷ್ಟ ವಯೋಮಿತಿಯನ್ನು ಅಭ್ಯರ್ಥಿಯು ಎಷ್ಟು ವರ್ಷಗಳ ಅವಧಿಗೆ ಆ ಹುದ್ದೆಯಲ್ಲಿ ಸೇವೆ ಸಲ್ಲಿಸುತ್ತಿರುವರೋ ಅಥವಾ ಹಿಂದೆ ಸಲ್ಲಿಸಿದ್ದಾರೋ ಅಷ್ಟು ವರ್ಷಗಳ ಅಥವಾ ಐದು ವರ್ಷಗಳ ಅವಧಿ ಅದರಲ್ಲಿ ಯಾವುದು ಕಡಿಮೆಯೋ ಅಷ್ಟು ವರ್ಷಗಳು

3. ಅಭ್ಯರ್ಥಿಗಳಿಗೆ ಕನ್ನಡ ಬಾಷಾ ಜ್ಞಾನದ ಅವಶ್ಯಕತೆ ಕಡ್ಡಾಯವಾಗಿರುತ್ತದೆ.
4. ಸರ್ಕಾರಿ ಇಲಾಖೆಯಲ್ಲಿ ಸೇವೆ ಸಲ್ಲಿಸುತ್ತಿರುವ ಅಭ್ಯರ್ಥಿಗಳು ಇಲಾಖಾ ಮುಖ್ಯಸ್ಥರಿಂದ ನಿರಾಕ್ಷೇಪಣಾ ಪತ್ರ ಪಡೆದುಕೊಂಡಿರಬೇಕು.
5. ಅಭ್ಯರ್ಥಿಗಳ ಆಯ್ಕೆ ಬಗ್ಗೆ ಶಿಫಾರಸ್ಸುಗಳನ್ನು ಮಾಡಿದರೆ ಅಂತಹವರ ಅರ್ಜಿಯನ್ನು ತಿರಸ್ಕರಿಸಲಾಗುವುದು
6. ಅರ್ಜಿದಾರರೊಡನೆ ಪತ್ರ ವ್ಯವಹಾರಕ್ಕೆ ಅವಕಾಶವಿರುವುದಿಲ್ಲ.
7. ಜಾತಿ ಮೀಸಲಾತಿಯಡಿಯಲ್ಲಿ ಆಯ್ಕೆಯಾದ ಅಭ್ಯರ್ಥಿಗಳು ಜಾತಿ ಪ್ರಮಾಣಪತ್ರದ ಬಗ್ಗೆ ಜಿಲ್ಲಾಧಿಕಾರಿಗಳು (ಅಧ್ಯಕ್ಷರು, ಜಾತಿ ಮತ್ತು ಆದಾಯ ಪರಿಶೀಲನಾ ಸಮಿತಿ) ರವರಿಂದ ಸಿಂಧುತ್ವ ಪ್ರಮಾಣಪತ್ರ ಪಡೆದ ನಂತರ ನೇಮಕಾತಿ ಆದೇಶ ನೀಡಲಾಗುವುದು.
8. ನೇಮಕಾತಿ ಬಗ್ಗೆ ಅಂತಿಮ ತೀರ್ಮಾನವನ್ನು ನೇಮಕಾತಿ ಪ್ರಾಧಿಕಾರಿಯಾದ ಜಿಲ್ಲಾಧಿಕಾರಿಗಳು, ಕೋಲಾರ ರವರು ಕಾಯ್ದಿರಿಸಿ ಕೊಂಡಿರುತ್ತಾರೆ.
9. **ಅರ್ಜಿ ಶುಲ್ಕದ ವಿವರ:**
    - ಪ.ಜಾತಿ/ ಪ.ಪಂಗಡ/ ಮಹಿಳಾ ಅಭ್ಯರ್ಥಿಗಳು **ರೂ. 100/–**
    - ಇತರರಿಗೆ **ರೂ. 200/–** ಗಳು ಮಾತ್ರ
10. ಆಯ್ಕೆಯನ್ನು **ಅಭ್ಯರ್ಥಿಯ ಮೆರಿಟ್** ಆಧಾರದ ಮೇಲೆ ಮಾತ್ರ ಪರಿಗಣಿಸಲಾಗುವುದು.
11. ಕಾಲೇಜಿನ ಪ್ರಾಂಶುಪಾಲರಿಂದ ಪಡೆದ ಒಂದು ನಡತೆ ಪ್ರಮಾಣಪತ್ರ ಹಾಗೂ ಸ್ಥಳೀಯ ಇಬ್ಬರು ಗಣ್ಯವ್ಯಕ್ತಿಗಳಿಂದ ಪಡೆದ 6 ತಿಂಗಳೊಳಗಿನ ಇತ್ತೀಚಿನ ನಡತೆ ಪ್ರಮಾಣಪತ್ರ ಲಗತ್ತಿಸಿರಬೇಕು.
12. **ಜಾತಿ / ಮೀಸಲಾತಿ ಪ್ರಮಾಣಪತ್ರಗಳು.**

    ಜಾತಿ ಮೀಸಲಾತಿ ಕೋರಬಯಸುವ ಪರಿಶಿಷ್ಟ ಜಾತಿ / ಪರಿಶಿಷ್ಟ ಪಂಗಡ ಅಭ್ಯರ್ಥಿಗಳು ನಮೂನೆ ಡಿ ರಲ್ಲಿ / ಪ್ರವರ್ಗ–1 ಅಭ್ಯರ್ಥಿಗಳು ನಮೂನೆ ಇ ನಲ್ಲಿ ಹಾಗೂ 2ಎ, 2ಬಿ, 3ಎ, 3ಬಿ ಅಭ್ಯರ್ಥಿಗಳು ನಮೂನೆ ಎಫ್ ನಲ್ಲಿ ಸಂಬಂಧಿತ ತಹಸೀಲ್ದಾರ್ ರವರಿಂದ ಪ್ರಮಾಣಪತ್ರವನ್ನು ಪಡೆದಿರಬೇಕು. ಈ ಪ್ರಮಾಣಪತ್ರವು ಈ ಹುದ್ದೆಗೆ ಅರ್ಜಿ ಸಲ್ಲಿಸಲು ನಿಗದಿಪಡಿಸಿರುವ ಕೊನೆಯ ದಿನಾಂಕದೊಳಗೆ ಪಡೆದಿರಬೇಕು ಹಾಗೂ ಚಾಲ್ತಿಯಲ್ಲಿರಬೇಕು ನಂತರ ಪಡೆದ ಪ್ರಮಾಣಪತ್ರಗಳನ್ನು ಪರಿಗಣಿಸುವುದಿಲ್ಲ.
13. **ಯೋಜನಾ ನಿರಾಶ್ರಿತರಾದ ಕುಟುಂಬದ ಅಭ್ಯರ್ಥಿಗಳು :**

    ಯೋಜನೆಗಳಿಂದ ನಿರಾಶ್ರಿತರಾದ ಕುಟುಂಬದ ಅಭ್ಯರ್ಥಿಗಳಿಗೆ ಮೀಸಲಿರಿಸಿದ ಹುದ್ದೆಗಳನ್ನು ಕೋರುವ ಅಭ್ಯರ್ಥಿಗಳು ಸಂಬಂಧಿಸಿದ ತಹಸೀಲ್ದಾರ್ ರವರಿಂದ ಸರ್ಕಾರದ ಅಧಿಸೂಚನೆ ಸಂಖ್ಯೆ ಡಿಪಿಎಆರ್ 23 ಎಸ್‌ಆರ್‌ಆರ್ 99 ದಿನಾಂಕ 23/11/2000 ರನ್ವಯ ಹಾಗೂ ಸರ್ಕಾರದ ಆದೇಶದ ಸಂಖ್ಯೆ ಸಿಆಸುಇ. 44 ಸೆಸೆನಿ 2001 ದಿನಾಂಕ 27/07/2001 ರಲ್ಲಿ ತಿಳಿಸಿರುವಂತೆ ನಿಗದಿತ ನಮೂನೆಯಲ್ಲಿ ದೃಢೀಕರಣ ಪತ್ರ ಪಡೆದುಕೊಂಡಿರಬೇಕು.

**14. ಮಾಜಿ ಸೈನಿಕರ ಕುಟುಂಬದ ಅಭ್ಯರ್ಥಿಗಳು :**

ಮಾಜಿ ಸೈನಿಕರು ಎನ್ನುವ ಬಗ್ಗೆ ಅಥವಾ ಭಾರತ ದೇಶದ ಒಕ್ಕೂಟದ ಸಶಸ್ತ್ರ ದಳದಲ್ಲಿ ಸೇವೆ ಸಲ್ಲಿಸುತ್ತಿರುವಾಗ ಕೊಲ್ಲಲ್ಪಟ್ಟ ಅಥವಾ ಶಾಶ್ವತವಾಗಿ ಅಂಗಹೀನರಾದ ವ್ಯಕ್ತಿಗಳ ಕುಟುಂಬದ ಸದಸ್ಯರು ಎಂಬ ಬಗ್ಗೆ ಸಕ್ಷಮ ಮಿಲಿಟರಿ ಅಧಿಕಾರಿಗಳಿಂದ/ ಸಕ್ಷಮ ಪ್ರಾಧಿಕಾರದಿಂದ ಪ್ರಮಾಣ ಪತ್ರವನ್ನು ಪಡೆದಿರಬೇಕು.

**15. ಅಂಗವಿಕಲ ಅಭ್ಯರ್ಥಿಗಳು :**

ಕರ್ನಾಟಕ ನಾಗರೀಕ ಸೇವಾ (ಸಾಮಾನ್ಯ ನೇಮಕಾತಿ) ನಿಯಮಗಳು 1977 ರ ನಿಯಮ 9(1–ಎ) ರ ಅನ್ವಯ ರಾಜ್ಯ ಸಿವಿಲ್ ಸೇವೆಯಲ್ಲಿನ ಗ್ರೂಪ್ ಸಿ ಹುದ್ದೆಗಳ ನೇರನೇಮಕಾತಿಯಲ್ಲಿ ಅಂಗವಿಕಲರಿಗೆ ಶೇ. 50ರಷ್ಟು ಸಮತಳ ಮೀಸಲಾತಿ ಕಲ್ಪಿಸಲಾಗಿದೆ.

ಸರ್ಕಾರದ ಆದೇಶ ಸಿಆಸುಇ 128 ಸೆನನಿ 2006 ದಿನಾಂಕ 1/8/2009 ರಂತೆ ನಿಗದಿಪಡಿಸಿದ ವಿವಿಧ ರೀತಿಯ ವೈಕಲ್ಯಗಳಿಗೆ ನಿಗದಿತ ಶೇಕಡವಾರು ಪ್ರಮಾಣದಲ್ಲಿ ಮೀಸಲಾತಿ ನೀಡಲಾಗುವುದು. ಸರ್ಕಾರದ ಅಧಿಕೃತ ಜ್ಞಾಪನ ಸಂಖ್ಯೆ ಸಿಆಸುಇ 115 ಸೆನನಿ 2005 ದಿ: 19/11/2005 ರಲ್ಲಿ ನಿಗದಿಪಡಿಸಿರುವ ನಮೂನೆಯಲ್ಲಿ ನಿಖರವಾದ ಅಂಗವಿಕಲತೆಯ ಬಗ್ಗೆ ಸಂಬಂಧಪಟ್ಟ ಜಿಲ್ಲಾ ಮಟ್ಟದ ವೈದ್ಯಕೀಯ ಮಂಡಳಿಯು ನೀಡುವ ಪ್ರಮಾಣಪತ್ರವನ್ನು ಪಡೆದು ಅದರ ದೃಢೀಕೃತ ಪ್ರತಿಯನ್ನು ಮೂಲ ದಾಖಲಾತಿ ಪರಿಶೀಲನಾ ಸಮಯದಲ್ಲಿ ಸಲ್ಲಿಸಬೇಕು.

ಸರ್ಕಾರಿ ಆದೇಶ ನಂ. ಡಿಪಿಎಆರ್ 07 ಸೇಸೇಅ 94 ದಿನಾಂಕ 13/9/1995 ರಲ್ಲಿ ನಿಗದಿಪಡಿಸಿರುವ ವೈದ್ಯಕೀಯ ಪ್ರಮಾಣಪತ್ರವನ್ನು ಸಕ್ಷಮ ವೈದ್ಯಾಧಿಕಾರಿಗಳಿಂದ ಪಡೆದಿರಬೇಕು ಮತ್ತು ಅಂಗವಿಕಲತೆ ಪ್ರಮಾಣವು ಕನಿಷ್ಟ ಶೇ. 40 ರಿಂದ ಗರಿಷ್ಟ 75 ಕ್ಕಿಂತ ಹೆಚ್ಚಾಗಿರಬಾರದು. ಈ ಪ್ರಮಾಣಪತ್ರವನ್ನು ಅರ್ಜಿ ಸ್ವೀಕರಿಸಲು ನಿಗದಿಪಡಿಸಿರುವ ಕಡೇಯ ದಿನಾಂಕದೊಳಗೆ ಅಭ್ಯರ್ಥಿಯು ಪಡೆದುಕೊಂಡಿರಬೇಕು.

**16. ಗ್ರಾಮೀಣ ಅಭ್ಯರ್ಥಿಗಳು:**

ಗ್ರಾಮೀಣ ಅಭ್ಯರ್ಥಿ ಎಂದರೆ ಒಂದು ಹುದ್ದೆಗಾಗಿ ನಿಯಮಿಸಲಾದ ಅರ್ಹತಾ ಪರೀಕ್ಷೆಯು ಎಸ್.ಎಸ್.ಎಲ್.ಸಿ. ಅಥವಾ ಉನ್ನತ ಪರೀಕ್ಷೆಯಾಗಿದ್ದಲ್ಲಿ 1ನೇ ತರಗತಿಯಿಂದ 10 ನೇ ತರಗತಿಯವರೆಗೆ ಗ್ರಾಮಾಂತರ ಪ್ರದೇಶಗಳಲ್ಲಿ ವ್ಯಾಸಂಗ ಮಾಡಿದ ಬಗ್ಗೆ ವ್ಯಾಸಂಗದ ಪ್ರಮಾಣಪತ್ರವನ್ನು ಸಂಬಂಧಪಟ್ಟ ಪ್ರಾಧಿಕಾರಿಯಿಂದ ಪಡೆದು ಕೊಂಡಿರಬೇಕು. ಗ್ರಾಮೀಣ ಮೀಸಲಾತಿಗೆ ಒಳಪಡುವ ಪ್ರದೇಶಗಳಲ್ಲಿ ವ್ಯಾಸಂಗ ಮಾಡಿ ಉತ್ತೀರ್ಣರಾಗಿರುವವರು ಈ ಮೀಸಲಾತಿ ಪಡೆಯಲು ಅರ್ಹರು. ಗ್ರಾಮೀಣ ಅಭ್ಯರ್ಥಿಗಳಿಗೆಂದು ಮೀಸಲಿರಿಸಿದ ಹುದ್ದೆಗಳನ್ನು ಕ್ಲೇಮ್ ಮಾಡುವ ಸಾಮಾನ್ಯ ಅರ್ಹತೆಯ ಅಭ್ಯರ್ಥಿಗಳು ನಮೂನೆ–2 ರ ಪ್ರಮಾಣ ಪತ್ರವಲ್ಲದೆ ಮೇಲುಸ್ತರಕ್ಕೆ ಸೇರಿಲ್ಲದಿರುವ ಬಗ್ಗೆ ನಮೂನೆ–1 ರಲ್ಲಿ ಪ್ರಮಾಣ ಪತ್ರವನ್ನು ಕಡ್ಡಾಯವಾಗಿ ಸಂಬಂಧಿಸಿದ ತಾಲ್ಲೂಕು ತಹಸೀಲ್ದಾರ್ ರವರಿಂದ ಪಡೆದುಕೊಂಡಿರಬೇಕು.

ಅಂತೆಯೇ ಗ್ರಾಮೀಣ ಮೀಸಲಾತಿ ಕೋರುವ ಪರಿಶಿಷ್ಟ ಜಾತಿ / ಪರಿಶಿಷ್ಟ ಪಂಗಡ, ಪ್ರವರ್ಗ–1, ಪವರ್ಗ–2ಎ, 2ಬಿ, 3ಎ, 3ಬಿ ಮೀಸಲಾತಿಗೆ ಸೇರಿದ ಅಭ್ಯರ್ಥಿಗಳು ಕಡ್ಡಾಯವಾಗಿ ಗ್ರಾಮೀಣ ಮೀಸಲಾತಿಯ ಪ್ರಮಾಣ ಪತ್ರವು ನಮೂನೆ–2 ರಲ್ಲಿ ನಿಗಧಿತ ಪ್ರಾಧಿಕಾರಿಗಳಿಂದ ಪಡೆದು ಕ್ಷೇತ್ರ ಶಿಕ್ಷಣಾಧಿಕಾರಿಯವರಿಂದ ಮೇಲು ರುಜು ಮತ್ತು ಮೊಹರು ಮಾಡಿಸಿಕೊಡು ಮೂಲ ದಾಖಲೆಗಳ ಪರಿಶೀಲನಾ ಸಮಯದಲ್ಲಿ ಸಲ್ಲಿಸಬೇಕು.

**17. ಕನ್ನಡ ಮಾಧ್ಯಮ ಅಭ್ಯರ್ಥಿಗಳು:**

ಸರ್ಕಾರದ ಅಧಿಸೂಚನೆ ಸಂ. ಡಿಪಿಎಆರ್ 71 ಎಸ್ಆರ್ಆರ್ 2001 ದಿನಾಂಕ 24–10–2002 ರಲ್ಲಿ ಹೊರಡಿಸಿದ ಕರ್ನಾಟಕ ಸರ್ಕಾರಿ ಸೇವಾ (ಸಾಮಾನ್ಯ ನೇಮಕಾತಿ) ನಿಯಮಗಳು 1977 ರ ನಿಯಮ 9(1)(ಸಿ) ರನ್ವಯ ಅಭ್ಯರ್ಥಿಯ 1 ರಿಂದ 10 ನೇ ತರಗತಿಯವರೆಗೆ ಕನ್ನಡ ಮಾಧ್ಯಮದಲ್ಲಿ ವ್ಯಾಸಂಗ ಮಾಡಿರುತ್ತಾರೆ ಎನ್ನುವ ಬಗ್ಗೆ ಸಂಬಂಧಪಟ್ಟ ಶಾಲೆಯ ಮುಖ್ಯೋಪಾಧ್ಯಾಯರ ಸಹಿ ಹಾಗೂ ಮೊಹರು ಪಡೆದ ಪ್ರಮಾಣ ಪತ್ರವನ್ನು ಸಂಬಂಧಪಟ್ಟ ಕ್ಷೇತ್ರಶಿಕ್ಷಣಾಧಿಕಾರಿಗಳಿಂದ ಮೇಲು ರುಜು ಮಾಡಿಸಿ ದೃಢೀಕೃತ ಪ್ರತಿಯನ್ನು ಮೂಲ ದಾಖಲಾತಿ ಪರಿಶೀಲನಾ ಸಮಯದಲ್ಲಿ ಸಲ್ಲಿಸಬೇಕು.

**18. ಅರ್ಹತಾ ಷರತ್ತುಗಳು :**

(ಅ) ಅರ್ಜಿದಾರರು ಭಾರತೀಯ ನಾಗರೀಕನಾಗಿರತಕ್ಕದ್ದು.

(ಆ) ಅಭ್ಯರ್ಥಿಯು ಮಾನಸಿಕವಾಗಿ ಮತ್ತು ದೈಹಿಕವಾಗಿ ಆರೋಗ್ಯವಂತನಾಗಿರಬೇಕು ಮತ್ತು ಅವರ ನೇಮಕಾತಿಯ ಕರ್ತವ್ಯಗಳ ದಕ್ಷ ನಿರ್ವಹಣೆಗೆ ಆತಂಕವನ್ನುಂಟು ಮಾಡುವ ಸಂಭವವಿರುವ ಯಾವುದೇ ದೈಹಿಕ ನ್ಯೂನತೆಯಿಂದ ಮುಕ್ತರಾಗಿರಬೇಕು.

(ಇ) ದೈಹಿಕವಾಗಿ/ಮಾನಸಿಕವಾಗಿ ಅನರ್ಹರಾಗಿದ್ದಾರೆಂಬುದಾಗಿ ವೈದ್ಯಕೀಯ ಮಂಡಳಿಯ ವರದಿಯ ಮೇಲೆ ಅಭ್ಯರ್ಥಿ ಹುದ್ದೆಗೆ ಅನರ್ಹರೆಂಬುದಾಗಿ ತಿರಸ್ಕರಿಸುವ ಪೂರ್ಣ ವಿವೇಚನೆಯನ್ನು ನೇಮಕಾತಿ ಪ್ರಾಧಿಕಾರ ಕಾಯ್ದಿರಿಸಿಕೊಂಡಿದೆ.

**19. ಪ್ರಮುಖವಾದ ಸೂಚನೆಗಳು.**

ಅಭ್ಯರ್ಥಿಗಳು ಕೆಳಕಂಡ ಪ್ರಮಾಣಪತ್ರಗಳನ್ನು ಮೂಲ ದಾಖಲಾತಿ ಪರಿಶೀಲನಾ ಸಮಯದಲ್ಲಿ ಸಲ್ಲಿಸಬೇಕು.

- ಹುದ್ದೆಗೆ ನಿಗದಿಪಡಿಸಲಾದ ವಿದ್ಯಾರ್ಹತೆಯ ಅಂಕಪಟ್ಟಿ ಪ್ರಮಾಣ ಪತ್ರ ಮತ್ತು ಕಂಪ್ಯೂಟರ್ ಜ್ಞಾನದ ಬಗ್ಗೆ ದಾಖಲೆ.
- ಜನ್ಮ ದಿನಾಂಕವನ್ನು ನಮೂದಿಸಿರುವ ಎಸ್.ಎಸ್.ಎಲ್.ಸಿ ಅಥವಾ ತತ್ಸಮಾನ ಪರೀಕ್ಷೆಯ ಪ್ರಮಾಣ ಪತ್ರ / ವರ್ಗಾವಣೆ ಪ್ರಮಾಣ ಪತ್ರವನ್ನು ಸಂಚಿತ ದಾಖಲೆಯ ಉದ್ಧೃತಭಾಗ (Cummulative Record)
- ಸೈನಿಕ ಸೇವೆಯಿಂದ ಬಿಡುಗಡೆಯಾದ / ಮುಕ್ತಿಹೊಂದಿದ ಬಗೆಗಿನ ಪ್ರಮಾಣ ಪತ್ರ (ಮೀಸಲಾತಿ ಕೋರಿದ್ದಲ್ಲಿ)
- ಪರಿಶಿಷ್ಟ ಜಾತಿ / ಪರಿಶಿಷ್ಟ ಪಂಗಡ, ಪ್ರವರ್ಗ–1, ಪವರ್ಗ–2ಎ, 2ಬಿ, 3ಎ, 3ಬಿ ಮೀಸಲಾತಿಯ ಪ್ರಮಾಣ ಪತ್ರಗಳು (ಮೀಸಲಾತಿ ಕೋರಿದ್ದಲ್ಲಿ)
- ಗ್ರಾಮೀಣ ಮೀಸಲಾತಿ ಪ್ರಮಾಣ ಪತ್ರ ನಮೂನೆ–1 ಮತ್ತು 2 ರಲ್ಲಿ (ಮೀಸಲಾತಿ ಕೋರಿದ್ದಲ್ಲಿ)
- ಕನ್ನಡ ಮಾಧ್ಯಮದಲ್ಲಿ ವ್ಯಾಸಂಗ ಮಾಡಿದ ಪ್ರಮಾಣ ಪತ್ರ (ಮೀಸಲಾತಿ ಕೋರಿದ್ದಲ್ಲಿ)
- ಯೋಜನೆಗಳಿಂದ ನಿರಾಶ್ರಿತರಾದ ಬಗ್ಗೆ ಪ್ರಮಾಣ ಪತ್ರ (ಮೀಸಲಾತಿ ಕೋರಿದ್ದಲ್ಲಿ)
- ವಿಧವೆಯಾಗಿದ್ದಲ್ಲಿ ಸಕ್ಷಮ ಪ್ರಾಧಿಕಾರದಿಂದ ಪಡೆದ ಪ್ರಮಾಣ ಪತ್ರ.
- ಅಂಗವಿಕಲ ಮೀಸಲಾತಿ ಪ್ರಮಾಣ ಪತ್ರ. (ಮೀಸಲಾತಿ ಕೋರಿದ್ದಲ್ಲಿ)

**20. ದುರ್ನಡತೆ:**

ಒಬ್ಬ ಅಭ್ಯರ್ಥಿಯು ನಕಲಿ ವ್ಯಕ್ತಿಯಾಗಿರುವನೆಂದು ಅಥವಾ ಖೋಟಾ ದಸ್ತಾವೇಜು ಅಥವಾ ತಿದ್ದಲಾದ ದಸ್ತಾವೇಜುಗಳನ್ನು ಸಲ್ಲಿಸಿರುವನೆಂದು ಅಥವಾ ತಪ್ಪು ಅಥವಾ ಸುಳ್ಳು ಹೇಳಿಕೆ ನೀಡಿರುವನೆಂದು ಅಥವಾ ವಾಸ್ತವಿಕ ಮಾಹಿತಿಯನ್ನು ಮರೆಮಾಚಿರುವನೆಂದು ಅಥವಾ ಅವರ ನೇಮಕಾತಿಯ ಸಂಬಂಧದಲ್ಲಿ ಯಾವುದೇ ಇತರ ಅಕ್ರಮ ಮತ್ತು ಅನುಚಿತ ಮಾರ್ಗವನ್ನು ಅನುಸರಿಸಿರುವುದು ಕಂಡು ಬಂದಲ್ಲಿ ಅವನು / ಅವಳು ಸ್ವಂತ: ಕ್ರಿಮಿನಲ್ ವ್ಯವಹರಣೆಗಳಿಗೆ ಮತ್ತು ಶಿಸ್ತು ಕ್ರಮಕ್ಕೆ ಒಳಪಡುವುದಲ್ಲದೆ, ಹುದ್ದೆಯ ಆಯ್ಕೆಯಿಂದ ಅಭ್ಯರ್ಥಿತ್ವವನ್ನು ರದ್ದುಪಡಿಸಲಾಗುವುದು.

**21. ಇತರೆ ಸೂಚನೆಗಳು :**

1. ಅಭ್ಯರ್ಥಿಗಳು ಆನ್‌ಲೈನ್‌ನಲ್ಲಿ ಪಡೆದ acknowledgement ಹಾಗೂ CHALLAN slip ನ್ನು ಬ್ಯಾಂಕ್‌ನಲ್ಲಿ ಪಾವತಿಸಿದ ನಂತರ ಅಭ್ಯರ್ಥಿಯ ಪ್ರತಿಯನ್ನು ಮಡಚುವುದಾಗಲೀ, ಹರಿಯುವುದಾಗಲೀ ಮಾಡದೇ ಹಾಳಾಗದಂತೆ ಎಚ್ಚರವಹಿಸತಕ್ಕದ್ದು.
2. ಸೇವೆಯಲ್ಲಿರುವ ಅಭ್ಯರ್ಥಿಗಳು ಅವರ ನೇಮಕಾತಿ ಪ್ರಾಧಿಕಾರದಿಂದ ನಿರಾಕ್ಷೇಪಣ ಪತ್ರ (No OBJECTION CERTIFICATE) ವನ್ನು ಪಡೆದು ಮೂಲ ದಾಖಲಾತಿ ಪರಿಶೀಲನಾ ಸಮಯದಲ್ಲಿ ಸಲ್ಲಿಸಬೇಕು.
3. ನೇಮಕಾತಿ ಬಗ್ಗೆ ಅಂತಿಮ ತೀರ್ಮಾನವನ್ನು ನೇಮಕಾತಿ ಪ್ರಾಧಿಕಾರದ ಅಧ್ಯಕ್ಷರಾದ ಜಿಲ್ಲಾಧಿಕಾರಿ, ಕೋಲಾರ ಜಿಲ್ಲೆ, ಕೋಲಾರ ಇವರು ಕಾಯ್ದಿರಿಸಿಕೊಂಡಿರುತ್ತಾರೆ.
4. ಕರ್ನಾಟಕ ಜನರಲ್ ಸರ್ವಿಸ್ (Revenue subordinated branch) (Cadre & Recruitment) (ತಿದ್ದುಪಡಿ) ನಿಯಮಗಳು 2008 ಮತ್ತು ಕರ್ನಾಟಕ ನಾಗರೀಕ ಸೇವಾ (ಸಾಮಾನ್ಯ ನೇಮಕಾತಿ) ನಿಯಮಗಳು 1977 ರ ಪ್ರಕಾರ ಅಭ್ಯರ್ಥಿಯನ್ನು ಅವರು ಪಿ.ಯು.ಸಿ. ಅಥವಾ ಸಿಬಿಎಸ್‌ಸಿ ಅಥವಾ ಐಸಿಎಸ್‌ಇ ನಡೆಸುವ 12 ನೇ ತರಗತಿ ಪರೀಕ್ಷೆಯಲ್ಲಿ ಪಡೆದ ಅಂಕಗಳ (on merit) ಅಧಾರದ ಮೇಲೆ ಅಯಾಯ ಮೀಸಲಾತಿ ಪ್ರವರ್ಗಕ್ಕೆ ಸಂಬಂಧಿಸಿದಂತೆ ಆಯ್ಕೆ ಮಾಡಲಾಗುವುದು.
5. ನೇಮಕಾತಿಯು ಸಂಪೂರ್ಣವಾಗಿ ಮೆರಿಟ್ ಮತ್ತು ಮೀಸಲಾತಿ ನಿಯಮಗಳನ್ವಯವೇ ನಡೆಯುತ್ತದೆ. ಯಾವುದೇ ರೀತಿಯ ಅಮಿಷಗಳಿಗೆ ಮೋಸಹೋಗದಿರಲು ಕೋರಿದೆ.
6. ಅಭ್ಯರ್ಥಿಯ ಹೆಸರು ಅಂತಿಮ ಆಯ್ಕೆ ಪಟ್ಟಿಯಲ್ಲಿ ಬಂದಿದೆ ಎಂಬುದರ ಆಧಾರದ ಮೇಲೆ ಅಭ್ಯರ್ಥಿಗೆ ನೇಮಕಾತಿಯಲ್ಲಿ ಯಾವುದೇ ಹಕ್ಕು ದೊರೆಯುವುದಿಲ್ಲ. ಆಯ್ಕೆಯ ಸಂಬಂಧವಾಗಿ ಈ ಕಛೇರಿಯೊಂದಿಗೆ ಯಾವುದೇ ಪತ್ರ ವ್ಯವಹಾರ ನಡೆಸಲು ಅಸ್ಪದ ಇರುವುದಿಲ್ಲ.

**ಅಧ್ಯಕ್ಷರು,**
**ಗ್ರಾಮಲೆಕ್ಕಾಧಿಕಾರಿಗಳ ನೇಮಕಾತಿ ಪ್ರಾಧಿಕಾರ**
**ಹಾಗೂ ಜಿಲ್ಲಾಧಿಕಾರಿಗಳು, ಕೋಲಾರ ಜಿಲ್ಲೆ, ಕೋಲಾರ.**

ಪಿ.ಆರ್. 104

## ಆರ್ಥಿಕ ಸಚಿವಾಲಯ

### ಅಧಿಸೂಚನೆ

**ಸಂಖ್ಯೆ : ಆಇ 98 ರಾಲೆಪ 2012, ಬೆಂಗಳೂರು, ದಿನಾಂಕ: 31–05–2012**

ಕರ್ನಾಟಕ ಗೆಜೆಟೆಡ್ ಪ್ರೊಬೇಷನರುಗಳ ನೇಮಕಾತಿ (ಸ್ಪರ್ಧಾತ್ಮಕ ಪರೀಕ್ಷೆಗಳ ಮೂಲಕ ನೇಮಕ) ನಿಯಮಗಳು 1997ರ ಅಡಿಯಲ್ಲಿ ಕರ್ನಾಟಕ ಲೋಕಸೇವಾ ಆಯೋಗವು ರಾಜ್ಯ ಲೆಕ್ಕಪತ್ರ ಇಲಾಖೆಯ ಗ್ರೂಪ್–ಎ ವೃಂದದ ಸಹಾಯಕ ನಿಯಂತ್ರಕರ ಹುದ್ದೆಗೆ ಅಭ್ಯರ್ಥಿಗಳನ್ನು ಆಯ್ಕೆ ಮಾಡಿ, ಆಯ್ಕೆ ಪಟ್ಟಿಯನ್ನು ಅಧಿಸೂಚನೆ ಸಂಖ್ಯೆ: ಇ(1)7797/2011–12 ಪಿಎಸ್‌ಸಿ ದಿ:15.3.2012ರ ರಾಜ್ಯಪತ್ರದಲ್ಲಿ ಪ್ರಕಟಿಸಿದೆ. ಈ ಆಯ್ಕೆ ಪಟ್ಟಿಯನ್ವಯ ಕೆಳಕಂಡ ಅಭ್ಯರ್ಥಿಗಳನ್ನು ರಾಜ್ಯ ಲೆಕ್ಕಪತ್ರ ಇಲಾಖೆಯಲ್ಲಿ ರೂ.28100–700–28800–800–33600–900–39000–1050–45300–1200–50100ರ ವೇತನ ಶ್ರೇಣಿಯ ಸಹಾಯಕ ನಿಯಂತ್ರಕರ ಹುದ್ದೆಗೆ ಪರಿವೀಕ್ಷಣೆ ಮೇಲೆ (On Probation) ನೇಮಕ ಮಾಡಲಾಗಿದೆ.

| ಕ್ರ ಸಂ. | ಆಯ್ಕೆ ಪಟ್ಟಿಯಲ್ಲಿನ ಕ್ರಮ ಸಂಖ್ಯೆ | ಅಭ್ಯರ್ಥಿಯ ಹೆಸರು ಮತ್ತು ವಿಳಾಸ<br>ಶ್ರೀ / ಶ್ರೀಮತಿ |
|---|---|---|
| 1 | 1 | ಅವಿನಾಶ್ ಜೆರಾಲ್ಡ್, ಎಂ.ದಾಸಾಪುರ, ಅಕ್ಕನಹಳ್ಳಿ ಪೋಸ್ಟ್, ನುಗ್ಗೇಹಳ್ಳಿ ಹೋಬಳಿ, ಚನ್ನರಾಯಪಟ್ಟಣ ತಾಲ್ಲೂಕು, ಹಾಸನ ಜಿಲ್ಲೆ –573131. |
| 2 | 2 | ಧರ್ಮಪಾಲ್ ಎಸ್. ನಂ.905, 1ನೇ ಮಹಡಿ, 3ನೇ ಕ್ರಾಸ್, 1ನೇ ಬ್ಲಾಕ್, ಕಲ್ಯಾಣ ನಗರ, ಬೆಂಗಳೂರು–560043. |
| 3 | 3 | ಅವಿನಾಶ್ ಕೆ.ಆರ್. ನಂ.42, 5ನೇ ಮೈನ್, 9ನೇ ಕ್ರಾಸ್, 3ನೇ ಫೇಸ್, ಗಿರಿನಗರ, ಬೆಂಗಳೂರು–560085. |
| 4 | 4 | ಮಧು ಡಿ.ಆರ್. S/o ರೇವಣ್ಣ ಸಿದ್ದಪ್ಪ, ದೇವಾಪುರ, ಹೊಸದುರ್ಗ ತಾಲ್ಲೂಕು, ಚಿತ್ರದುರ್ಗ–577527 |
| 5 | 6 | ಸುಬೇಶ ಎಸ್. ನಂ.133/1, ಗಂಗಮ್ಮ ಲೇಔಟ್, ಹೆಬ್ಬಾಳ ಗುಡ್ಡದಹಳ್ಳಿ ರೈಲ್ವೆ ಟ್ರಾಕ್ ಹತ್ತಿರ, ಆರ್.ಟಿ.ನಗರ ಪೋಸ್ಟ್, ಬೆಂಗಳೂರು–560032 |
| 6 | 7 | ರಾಜು ಎಸ್.ಕೆ. ಅಗಲೇರಿ ರಸ್ತೆ, ಸಾಲಿಗ್ರಾಮ, ಕೆ.ಆರ್.ನಗರ ತಾಲ್ಲೂಕು, ಮೈಸೂರು ಜಿಲ್ಲೆ–571604 |
| 7 | 8 | ಪ್ರಶಾಂತ ನಾಯಕ ಜಿ. S/o ಗುರುವಯ್ಯ ಎನ್.ಜಿ., ಬೆಸ್ಕಾಂ ನೌಕರ, ವಿಠಲ ನಗರ, ಚಳ್ಳಕೆರೆ–577522. |
| 8 | 9 | ಸುಬ್ಬರಾಮಯ್ಯ ಜೆ.ಎಸ್. ಹೊಲ್ಲಂಬಳ್ಳಿ ವಿಲೇಜ್, ಶಾಪುರ ಪೋಸ್ಟ್, ಕೋಲಾರ ತಾಲ್ಲೂಕು, ಕೋಲಾರ–563101 |
| 9 | 12 | ರೇಖ ಕೆ.ಎಸ್. ನಂ.239, 16ನೇ ಮೈನ್, 3ನೇ ಸೆಕ್ಟರ್, ಹೆಚ್.ಎಸ್.ಆರ್. ಲೇಔಟ್, ಬೆಂಗಳೂರು–560034. |
| 10 | 13 | ವಾಣಿ ಎನ್. ನಂ.984 ಬಿ ಲೇಔಟ್ ಎಸ್.ಎಸ್. ನಗರ, ಬನ್ನಿಮಂಟಪ್, ಮೈಸೂರು–570015 |
| 11 | 15 | ಗುರುಬಸವೇ ಗೌಡ ಎ.ವಿ. ನಂ.361, 2ನೇ ಮಹಡಿ, 10ನೇ ಕ್ರಾಸ್, ಕುವೆಂಪು ನಗರ, ಹಾಸನ–573201. |
| 12 | 17 | ಪ್ರಿಯಾಂಕ ನೀಷ್ಮಾ ಡಿ ಕೋಸ್ಟ, ಪ್ರೇರಣ, ನಂ.393, ಮದರ್ ತೆರೇಸ ರಸ್ತೆ, ವಿದ್ಯಾನಗರ, ಹಾಸನ–573201. |
| 13 | 18 | ಭಾವನ ಭಟ್ ಎಸ್.ಎ. ನಂ.13/1, ರಂಗರಾವ್ ಪ್ಯಾರಲಲ್ ರಸ್ತೆ, ಶಂಕರಪುರಂ, ಬೆಂಗಳೂರು–560004. |
| 14 | 19 | ರಾಧಿಕ ಜಿ. 1226, 2ನೇ ಮೈನ್, 3ನೇ ಸ್ಟೇಜ್, ಬಿ.ಇ.ಎಂ.ಎಲ್. ಲೇಔಟ್, ಆರ್.ಆರ್.ನಗರ, ಬೆಂಗಳೂರು–560098. |
| 15 | 20 | ಕವಿತಾ ಡಿ.ಬಿ. ರುದ್ರ ಕುಮಾರ್ ವೈ.ಎಸ್. ಶ್ರೀ ಐಯ್ಯಂಗಾರ್ ಬೇಕರಿ, ನಂ.88 ಇ, 13ನೇ ಕ್ರಾಸ್,<br>ಅಯ್ಯಪ್ಪ ಸ್ವಾಮಿ ದೇವಸ್ಥಾನದ ಎದುರು, ಮಹಾಲಕ್ಷ್ಮಿ ಲೇಔಟ್, ಬೆಂಗಳೂರು–560086. |
| 16 | 21 | ಜ್ಯೋತಿ ಡಿ.ಕುಂದರ್, ಗುಜ್ಜಾರಬೆಟ್ಟು, ಪುಡುಕೋನ್ಸೆ ಹಳ್ಳಿ, ಕೆಮ್ಮಣ್ಣು ಪೋಸ್ಟ್, ಉಡುಪಿ–576115 |
| 17 | 22 | ಶ್ವೇತ ಹೆಚ್.ವಿ. D/o ಹೆಚ್.ಎನ್.ವಾಸಣ್ಣ, 1771, ಪಂಚಮುಖಿ, ಟೆಲಿಫೋನ್ ಎಕ್ಸ್‌ಚೇಂಜ್ ಹಿಂಭಾಗ, ಸಂಕ್ರಾಂತಿ ಸರ್ಕಲ್, ಹೆಬ್ಬಾಳ 2ನೇ ಹಂತ, ಮೈಸೂರು–570017. |
| 18 | 23 | ಗಾಯತ್ರಿ ಬಿ. ಪೇಟೆ ಗಂಗಮಾತಾ ಬೀದಿ, ಕೆಳಗಾಲಕೇರಿ, ಮಳವಳ್ಳಿ ಟೌನ್, ಮಂಡ್ಯ ಜಿಲ್ಲೆ–571430 |
| 19 | 24 | ದೇವಕಿ ಎನ್.ಕೆ. ಹೇಮನಹಳ್ಳಿ ವಿಲೇಜ್, ಮುರಕನಹಳ್ಳಿ ಪೋಸ್ಟ್, ಕಸಬಾ ಹೋಬಳಿ, ಕೆ.ಆರ್.ಪೇಟೆ ತಾ; ಮಂಡ್ಯ ಜಿಲ್ಲೆ, ಕೃಷ್ಣರಾಜಪೇಟೆ–571426 |
| 20 | 25 | ರಾಮಣ್ಣ ಅಥಣಿ, ಎ/ಪಿ ಕೆಹೆಚ್‌ಪಿಎಸ್ ನದಿ ಇಂಗಾಲಗಾಂವ್ ತಾ: ಅಥಣಿ, ಬೆಳಗಾಂ ಜಿಲ್ಲೆ, ಅಥಣಿ–591304 |
| 21 | 26 | ಶ್ರೀಲಕ್ಷ್ಮಿ ಟಿ.ಕೆ. C/o ಚಿನ್ನಕೋಟಯ್ಯ ಕಾಂಪೌಂಡ್, ಎಸ್.ಎಸ್.ಪುರಂ, 11ನೇ ಕ್ರಾಸ್, ತುಮಕೂರು–572102 |

| ಕ್ರ. ಸಂ. | ಆಯ್ಕೆ ಪಟ್ಟಿಯಲ್ಲಿನ ಕ್ರಮ ಸಂಖ್ಯೆ | ಅಭ್ಯರ್ಥಿಯ ಹೆಸರು ಮತ್ತು ವಿಳಾಸ ಶ್ರೀ / ಶ್ರೀಮತಿ |
|---|---|---|
| 22 | 27 | ಮುತ್ತರಾಜು ಎಲ್. ಬುಯ್ಯನದೊಡ್ಡಿ ವಿಲೇಜ್, ಎನ್.ಕೆ.ಹಳ್ಳಿ ಪೋಸ್ಟ್, ಹಲಗುರ್ ಹೋಬಳಿ, ಮಳವಳ್ಳಿ ತಾ: ಮಂಡ್ಯ ಜಿಲ್ಲೆ–571421 |
| 23 | 28 | ವರದರಾಜು ಎನ್.ಎಸ್. S/o ಸಿದ್ದಬಸವಯ್ಯ, ನಿವೃತ್ತ ಲೆಕ್ಚರರ್, ವಿಜಯನಗರ ಬಡಾವಣೆ, ಹುಳಿಯಾರ್, ಸಿ.ಎನ್.ಹಳ್ಳಿ ತಾ: ತುಮಕೂರು ಜಿಲ್ಲೆ, ಹುಳಿಯಾರ್–572218. |
| 24 | 29 | ಲಲಿತಾ ಕೆ. D/o ಕೃಷ್ಣಪ್ಪ ಸಿ, C/o ಜಯಮ್ಮ ಟೀಚರ್, ಮೋತಿಲಾಲ್ ರಸ್ತೆ, ಶ್ರೀನಿವಾಸಪುರ ತಾ: ಕೋಲಾರ ಜಿಲ್ಲೆ, ಶ್ರೀನಿವಾಸಪುರ–563135. |
| 25 | 30 | ಲಕ್ಷ್ಮಿ ಸಾಗರ್ ಎನ್.ಕೆ. C/o ಸಿದ್ದರಾಮು ಕೆ.ಪಿ, ಶ್ರೀ ಕೆ.ಬಿ.ಪೇಂಟ್ಸ್, ರಾಯರದೊಡ್ಡಿ ಸರ್ಕಲ್, ಮಾಗಡಿ ರಸ್ತೆ, ರಾಮನಗರಂ ತಾಲ್ಲೂಕು/ಜಿಲ್ಲೆ, ರಾಮನಗರಂ–571511 |
| 26 | 31 | ಪದ್ಮಿನಿ ಎಂ.ಎಸ್. ನಂ.1700, ಹುಲ್ಲಿನ ಬೀದಿ, 1ನೇ ಕ್ರಾಸ್, ಕೆ.ಆರ್.ಮೊಹಲ್ಲಾ, ಮೈಸೂರು–570004. |
| 27 | 36 | ಶ್ರೀನಿವಾಸಲು ಆರ್. ಅಪ್ಪಣ್ಣ ಬಿಲ್ಡಿಂಗ್, ಡಾ:ಅಂಬೇಡ್ಕರ್ ನಗರ, ಬಂಗಾರಪೇಟೆ ರಸ್ತೆ, ಕೋಲಾರ–563101 |
| 28 | 41 | ವಿಕ್ರಂ ಆರ್.ನಾಯಕ್, C/o ಆರ್.ಕೆ.ನಾಯಕ್ ಡಿ.ಎಸ್.ಪಿ, ನಂ.64, ಬಸವ ನಿಲಯ, ಅಂಬಾದೇವಿ ದೇವಸ್ಥಾನದ ಹತ್ತಿರ, ಗಚ್ಚಿನಕಟ್ಟಿ ಕಾಲೋನಿ, ಬಿಜಾಪುರ–586103. |
| 29 | 43 | ಅಮೀನಾಸಾಬ್, ಎ.ಎಂ.ಅತ್ತರ್ ಎಟಿ/ಪೋಸ್ಟ್, ಕೂಡಲಸಂಗಮ ತಾ:, ಹುನಗುಂದ ಜಿಲ್ಲೆ, ಬಾಗಲಕೋಟೆ, ಕೂಡಲಸಂಗಮ–587115. |
| 30 | 45 | ಮಂಜುಳ ಹೆಚ್.ಪಿ. ನಂ. ಎ 5, 2ನೇ ಮಹಡಿ, ಜಾಲಹಳ್ಳಿ ಪೋಲೀಸ್ ಕಾಲೋನಿ, ಹೆಚ್.ಎಂ.ಟಿ. ಪೋಸ್ಟ್, ಬೆಂಗಳೂರು–560013. |
| 31 | 46 | ಪರಶುರಾಂ ದುಡಗುಂಟಿ, AT.PO. ಅಂಕಲಗಿ, ಗೋಕಾಕ್ ತಾ: ಬೆಳಗಾಂ ಜಿಲ್ಲೆ, ಗೋಕಾಕ್–591101 |
| 32 | 47 | ಮಂಜುನಾಥ್ ಹೆಗ್ಡೆ, ನಂ.549, 14ನೇ ಕ್ರಾಸ್, ಶ್ರೀರಾಂ ಪುರ, 2ನೇ ಹಂತ, ಮೈಸೂರು, ಮೈಸೂರು–570023 |
| 33 | 48 | ಮಹಾಂತೇಶ್ ಚಿವಟಗುಂಡಿ, C/o ದೀಪಕ್ ಗವಲಿ, ಸಿಸಿಬಿ–45, ಸರ್ವೋದಯ ಕಾಲೋನಿ, ಹಿಂದವಾಡಿ, ಬೆಳಗಾಂ–590011 |
| 34 | 49 | ರವೀಶಾ ಕೆ.ಎಲ್. ಸಬ್ ಇನ್ಸ್‌ಪೆಕ್ಟರ್ ಆಫ್ ಪೋಲೀಸ್, ಟ್ರಾಫಿಕ್ ಪೋಲೀಸ್ ಸ್ಟೇಷನ್, ಉಡುಪಿ–576101 |

ಕರ್ನಾಟಕ ಗೆಜೆಟೆಡ್ ಪ್ರೊಬೇಷನರುಗಳ ನೇಮಕಾತಿ (ಸ್ಪರ್ಧಾತ್ಮಕ ಪರೀಕ್ಷೆಗಳ ಮೂಲಕ ನೇಮಕ) ನಿಯಮಗಳು 1997ರ ನಿಯಮ 11(iii)ರನ್ವಯ ಆಯ್ಕೆಯಾದ ಅಭ್ಯರ್ಥಿಗಳ ಜೇಷ್ಠತೆಯು ಆಯ್ಕೆ ಪಟ್ಟಿಯಲ್ಲಿರುವ ಜೇಷ್ಠತೆಯಂತೆ ಇರುತ್ತದೆ.

ಆಯ್ಕೆ ಪಟ್ಟಿಯಲ್ಲಿರುವ ಮೇಲ್ಕಂಡ ಅಭ್ಯರ್ಥಿಗಳ ನೇಮಕಾತಿಯು ಕರ್ನಾಟಕ ಆಡಳಿತ ನ್ಯಾಯಮಂಡಳಿಯಲ್ಲಿನ ಅರ್ಜಿ ಸಂಖ್ಯೆ:1772/2010, 5130/2010, 3310–45/2011, 3456–58/2011, 3547/2011, 3642/2011, 3840–59/2011, 4405/2011 ಮತ್ತು 609–610/2012 ಗಳಲ್ಲಾಗುವ ಅಂತಿಮ ತೀರ್ಪಿಗೆ ಒಳಪಟ್ಟಿರುತ್ತದೆ.

ಈ ಎಲ್ಲಾ ಅಭ್ಯರ್ಥಿಗಳು ಎರಡು ವರ್ಷಗಳ ಅವಧಿಯಲ್ಲಿ ಪರೀಕ್ಷಾರ್ಥ ತರಬೇತಿಯಲ್ಲಿರುತ್ತಾರೆ. ಈ ಅವಧಿಯಲ್ಲಿ 1974ರ ಕರ್ನಾಟಕ ಸಿವಿಲ್ ಸೇವೆಗಳು (ಸೇವಾ ಮತ್ತು ಕನ್ನಡ ಭಾಷಾ ಪರೀಕ್ಷೆಗಳು) ನಿಯಮಾವಳಿಯಲ್ಲಿ ನಿಗದಿಪಡಿಸಿರುವ ಎಲ್ಲಾ ಇಲಾಖಾ ಪರೀಕ್ಷೆಗಳಲ್ಲಿ ಉತ್ತೀರ್ಣರಾಗಬೇಕು. ರಾಜ್ಯ ಲೆಕ್ಕ ಪತ್ರ ಇಲಾಖೆಯ ವೃಂದ ಮತ್ತು ನೇಮಕಾತಿ ನಿಯಮಗಳಲ್ಲಿ ನಿಗದಿಪಡಿಸಿದ ತರಬೇತಿ ಪಡೆಯುವುದು ಕಡ್ಡಾಯವಾಗಿದೆ. ಪರೀಕ್ಷಾರ್ಥ ಅವಧಿಯನ್ನು ತೃಪ್ತಿಕರವಾಗಿ ಪೂರೈಸಬೇಕು.

ಈ ಅಭ್ಯರ್ಥಿಗಳ ನೇಮಕಾತಿ ಮತ್ತು ಸೇವಾ ಷರತ್ತುಗಳು ಆಗಿಂದಾಗ್ಗೆ ಜಾರಿಯಲ್ಲಿರುವ ನಿಯಮ / ಆದೇಶದ ಅಧೀನಕ್ಕೆ ಒಳಪಟ್ಟಿರುತ್ತವೆ.

ಈ ಅಧಿಸೂಚನೆಯನ್ನು ನೊಂದಾಯಿತ ಅಂಚೆ ಮೂಲಕ ರವಾನಿಸಿದ್ದು, ಅಭ್ಯರ್ಥಿಗಳು ನೇಮಕಾತಿ ಆದೇಶ ತಲುಪಿದ ದಿನಾಂಕದಿಂದ 15 ದಿನಗಳೊಳಗೆ ನಿಯಂತ್ರಕರು, ರಾಜ್ಯ ಲೆಕ್ಕಪತ್ರ ಇಲಾಖೆ, ಕಾವೇರಿ ಭವನ, 6ನೇ ಮಹಡಿ, ಕೆಂಪೇಗೌಡ ರಸ್ತೆ, ಬೆಂಗಳೂರು–560009, ಇವರಲ್ಲಿ ಕರ್ತವ್ಯಕ್ಕೆ ಹಾಜರಾಗತಕ್ಕದ್ದು. ಇದಕ್ಕೆ ತಪ್ಪಿದಲ್ಲಿ ಅಭ್ಯರ್ಥಿಯ ನೇಮಕಾತಿಯು ರದ್ದಾಗುವುದು.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

**ಬಿ.ಎಲ್. ರಮೇಶ,**
ಸರ್ಕಾರದ ಅಧೀನ ಕಾರ್ಯದರ್ಶಿ,
ಆರ್ಥಿಕ ಇಲಾಖೆ (ಆಡಳಿತ & ಮುಂಗಡ)

**ಪಿ.ಆರ್. 102**